RNI No. **KARBIL/2001/47147**



# ಕರ್ನಾಟಕ ರಾಜ್ಯಪತ್ರ

**ಅಧಿಕೃತವಾಗಿ ಪ್ರಕಟಿಸಲಾದುದು**

| ಸಂಪುಟ ೧೪೮<br>**Volume 148** | ಬೆಂಗಳೂರು, ಗುರುವಾರ, ಜನವರಿ ೩, ೨೦೧೩ (ಪುಷ್ಯ ೧೩, ಶಕ ವರ್ಷ ೧೯೩೪)<br>**Bangalore, Thursday, January 3, 2013 (Pushya 13, Shaka Varsha 1934)** | ಸಂಚಿಕೆ ೧<br>**Issue 1** |
|---|---|---|

## ಭಾಗ – ೧

## ರಾಜ್ಯ ಸರ್ಕಾರದ ಮುಖ್ಯ ಆದೇಶಗಳು ಹಾಗೂ ಸುತ್ತೋಲೆ ಮುಂತಾದ ಎಲ್ಲಾ ಇಲಾಖೆಗಳಿಗೂ ಸಂಬಂಧಿಸಿದ ಆದೇಶಗಳು

### ಆಹಾರ, ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಸಚಿವಾಲಯ

### ಸುತ್ತೋಲೆ

**ಸಂಖ್ಯೆ: ಅನಾಸ 176 ಡಿಆರ್‌ಎ 2010 ಬೆಂಗಳೂರು, 3ನೇ ಅಕ್ಟೋಬರ್, 2012**

**ವಿಷಯ :** ಕರ್ನಾಟಕ ಅಗತ್ಯ ವಸ್ತುಗಳ ಪರವಾನಗಿ ಆದೇಶ 1986ರ ಅಡಿ ನ್ಯಾಯಬೆಲೆ ಅಂಗಡಿ/ಚಿಲ್ಲರೆ ಸೀಮೆಎಣ್ಣೆ ಅಂಗಡಿಗೆ ಪರವಾನಗಿ ಪಡೆದು, ಕರ್ನಾಟಕ ಅಗತ್ಯ ವಸ್ತುಗಳ (ಸಾವಿಪ) ನಿಯಂತ್ರಣ ಆದೇಶ 1992ರ ಅಡಿ ನ್ಯಾಯಬೆಲೆ ಅಂಗಡಿ/ಚಿಲ್ಲರೆ ಸೀಮೆಎಣ್ಣೆ ಪ್ರಾಧಿಕಾರಗಳ ಮಂಜೂರಾತಿ ಅಥವಾ ನವೀಕರಣಕ್ಕೆ ಅರ್ಜಿ ಸಲ್ಲಿಸಿದಾಗ ತೆಗೆದುಕೊಳ್ಳಬೇಕಾದ ಕ್ರಮಗಳ ಬಗ್ಗೆ.

**ಉಲ್ಲೇಖ :** ಆಯುಕ್ತರು, ಆಹಾರ, ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಇಲಾಖೆ ಅವರ ಪತ್ರ ಸಂ. ಸಿಎಫ್‌ಎಸ್. ಪಿಡಿ.ಸೀಎ: 434/2006-07, ದಿನಾಂಕ : 02-09-2010.

ಕರ್ನಾಟಕ ಅಗತ್ಯ ವಸ್ತುಗಳ (ಸಾ.ವಿ.ಪ) ನಿಯಂತ್ರಣ ಆದೇಶ 1992 ಜಾರಿಗೆ ಬರುವ ಮುನ್ನ ನ್ಯಾಯಬೆಲೆ ಅಂಗಡಿ/ಚಿಲ್ಲರೆ ಸೀಮೆಎಣ್ಣೆ ಅಂಗಡಿಗಳಿಗೆ ಪರವಾನಗಿಯನ್ನು ಕರ್ನಾಟಕ ಅಗತ್ಯ ವಸ್ತುಗಳ ಪರವಾನಗಿ ಆದೇಶ 1986 (ಇನ್ನು ಮುಂದೆ ಸಂಕ್ಷಿಪ್ತವಾಗಿ '1986ರ ಪರವಾನಗಿ ಆದೇಶ' ಎಂದು ಕರೆಯಲಾಗುವುದು) ರಡಿ ನೀಡಲಾಗುತ್ತಿತ್ತು. 1992ರ ಕರ್ನಾಟಕ ಅಗತ್ಯ ವಸ್ತುಗಳ (ಸಾ.ವಿ.ಪ) ನಿಯಂತ್ರಣ ಆದೇಶ (ಇನ್ನು ಮುಂದೆ ಸಂಕ್ಷಿಪ್ತವಾಗಿ '1992ರ ನಿಯಂತ್ರಣ ಆದೇಶ' ಎಂದು ಕರೆಯಲಾಗುವುದು) ಜಾರಿಗೆ ಬಂದ ನಂತರ, ನ್ಯಾಯಬೆಲೆ ಅಂಗಡಿ ನಡೆಸುವವರು ಮತ್ತು ಸೀಮೆಎಣ್ಣೆ ವಿತರಕರು ಸದರಿ ಆದೇಶದಡಿ ಪ್ರಾಧಿಕಾರವನ್ನೂ ಹಾಗೂ 1986ರ ಪರವಾನಗಿ ಆದೇಶದನ್ವಯ ಪರವಾನಗಿಯನ್ನೂ ಹೊಂದುವುದು ಅಗತ್ಯವಾಗಿರುತ್ತದೆ.

1986ರ ಪರವಾನಗಿ ಆದೇಶದಡಿ ಪರವಾನಗಿಯನ್ನು ಮಾತ್ರ ಪಡೆದು ವ್ಯವಹರಿಸುತ್ತಿರುವ, ಆದರೆ 1992ರ ನಿಯಂತ್ರಣ ಆದೇಶದಡಿ ಪ್ರಾಧಿಕಾರ ಪಡೆಯದೇ ಅಥವಾ ಪ್ರಾಧಿಕಾರ ಪಡೆದಿದ್ದರೂ, ಮುಂದಿನ ಅವಧಿಗೆ ನವೀಕರಿಸಿಕೊಳ್ಳದ ಕೆಲವು ಪ್ರಕರಣಗಳಲ್ಲಿ ಪರವಾನಗಿಗಳನ್ನು ಏಕಾಏಕಿ ರದ್ದುಗೊಳಿಸಿದರೆ ಪಡಿತರ ವಿತರಣೆಯಲ್ಲಿ ಗೊಂದಲ ಉಂಟಾಗುತ್ತದೆಂದು, ಅಂತಹ ಪರವಾನಗಿದಾರರುಗಳಿಗೆ ದಂಡವಿಧಿಸಿ 1992ರ ನಿಯಂತ್ರಣ ಆದೇಶದಡಿ ಪ್ರಾಧಿಕಾರ ಮಂಜೂರು ಮಾಡಲು ಅಥವಾ ನವೀಕರಿಸಲು ಸೂಕ್ತ ಆದೇಶ ನೀಡುವಂತೆ ಓದಲಾದ ಪತ್ರದಲ್ಲಿ ಆಯುಕ್ತರು, ಆಹಾರ, ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಇಲಾಖೆ ಅವರು ಕೋರಿರುತ್ತಾರೆ.

ಮೇಲೆ ವಿವರಿಸಿದ ಅಂಶಗಳ ಹಿನ್ನೆಲೆಯಲ್ಲಿ, ಈಗಾಗಲೇ 1986ರ ಪರವಾನಗಿ ಆದೇಶದಡಿ ಆಹಾರಧಾನ್ಯ/ಸೀಮೆಎಣ್ಣೆ ವಹಿವಾಟು ನಡೆಸಲು ಪರವಾನಗಿ ಹೊಂದಿರುವವರಿಗೆ, 1992ರ ನಿಯಂತ್ರಣ ಆದೇಶದಡಿ ಪ್ರಾಧಿಕಾರ ಮಂಜೂರು ಮಾಡಲು ಅಥವಾ ನವೀಕರಿಸಲು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಸರ್ಕಾರದ ಮಂಜೂರಾತಿ ನೀಡಿದೆ.

i) ಸರ್ಕಾರದ ಆದೇಶ ಸಂಖ್ಯೆ : ಆನಾಸ 11 ಎಫ್‌ಸಿಎಸ್ 2012, ದಿನಾಂಕ : 26ನೇ ಮಾರ್ಚ್ 2012 ಮತ್ತು ಸರ್ಕಾರದ ಆದೇಶ ಸಂಖ್ಯೆ : ಆನಾಸ 36 ಆನಾಸ 2011, ದಿನಾಂಕ : 18ನೇ ಜೂನ್ 2012ರಲ್ಲಿನ ಅಂಶಗಳನ್ನು ಕಡ್ಡಾಯವಾಗಿ ಗಣನೆಗೆ ತೆಗೆದುಕೊಂಡು, ಪರಿಶೀಲಿಸಿ ಎಲ್ಲಾ ಅಂಶಗಳನ್ನು ಪಾಲಿಸಲಾಗಿದ್ದರೆ ಮಾತ್ರ ಪ್ರಾಧಿಕಾರ ಮಂಜೂರು ಮಾಡುವುದು ಅಥವಾ ನವೀಕರಿಸುವುದು

ii) 1992ರ ನಿಯಂತ್ರಣ ಆದೇಶದಡಿ ಪ್ರಾಧಿಕಾರ ಮಂಜೂರು ಅಥವಾ ನವೀಕರಿಸುವ ಮುನ್ನ ನ್ಯಾಯಬೆಲೆ ಅಂಗಡಿಗಳ ಅಥವಾ ಚಿಲ್ಲರೆ ಸೀಮೆಎಣ್ಣೆ ಅಂಗಡಿ ಪ್ರಾಧಿಕಾರಗಳ Web based database ಅನ್ನು ಸಿದ್ದಪಡಿಸಿ, ಅದರಲ್ಲಿಯೇ ಪ್ರಾಧಿಕಾರ ಮಂಜೂರು ಮತ್ತು ನವೀಕರಣವನ್ನು ನಿರ್ವಹಿಸತಕ್ಕದ್ದು.

iii) ಪರವಾನಗಿ ಪಡೆದ ನ್ಯಾಯಬೆಲೆ ಅಂಗಡಿ/ಚಿಲ್ಲರೆ ಸೀಮೆಎಣ್ಣೆ ಅಂಗಡಿ ವಿರುದ್ಧ ಯಾವುದೇ ನ್ಯಾಯಾಲಯದಲ್ಲಿ/ಸಕ್ಷಮ ಪ್ರಾಧಿಕಾರಗಳಲ್ಲಿ ದೂರು ದಾಖಲಾಗಿ, ವಿಲೇ ಬಾಕಿ ಇದ್ದಲ್ಲಿ ಅಥವಾ ಆರೋಪವು ಸಾಬೀತಾಗಿ ಶಿಕ್ಷೆ/ದಂಡ ವಿಧಿಸಿದ್ದಲ್ಲಿ ಅಂತಹವರಿಗೆ ಪ್ರಾಧಿಕಾರ ಮಂಜೂರು ಮಾಡತಕ್ಕದ್ದಲ್ಲ ಅಥವಾ ನವೀಕರಿಸತಕ್ಕದಲ್ಲ.

iv) ಯಾವುದೇ ಕಾರಣಕ್ಕೆ ಈಗಾಗಲೇ ರದ್ದಾಗಿರುವ ನ್ಯಾಯಬೆಲೆ ಅಂಗಡಿ/ಚಿಲ್ಲರೆ ಸೀಮೇಎಣ್ಣೆ ಪರವಾನಗಿಗಳಿಗೆ ಪ್ರಾಧಿಕಾರವನ್ನು ಮಂಜೂರು ಮಾಡತಕ್ಕದ್ದಲ್ಲ ಅಥವಾ ನವೀಕರಿಸತಕ್ಕದ್ದಲ್ಲ.

v) ಕರ್ನಾಟಕ ಅಗತ್ಯ ವಸ್ತುಗಳ ಪರವಾನಗಿ ಆದೇಶ 1986ರ ಅಡಿ ಪರವಾನಗಿ ನವೀಕರಣಕ್ಕೆ ಪ್ರತಿ ವರ್ಷಕ್ಕೆ clause-5 ರ ಕೆಳಗೆ ನಿಗಧಿಪಡಿಸಿದ ಮೊತ್ತವನ್ನು ಸಂಗ್ರಹಿಸಬೇಕು ಮತ್ತು ಕರ್ನಾಟಕ ಅಗತ್ಯ ವಸ್ತುಗಳ (ಸಾ.ವಿ.ಪ) ನಿಯಂತ್ರಣ ಆದೇಶ 1992ರ ಅಡಿ ಪ್ರಾಧಿಕಾರ ಮಂಜೂರು ಮಾಡಲು ಅಥವಾ ನವೀಕರಿಸಲು ಪ್ರತಿ ವರ್ಷಕ್ಕೆ ಸದರಿ ಆದೇಶದ clause-7 ರಡಿ ನಿಗಧಿಪಡಿಸಿದ ಮೊತ್ತವನ್ನು ಸಂಗ್ರಹಿಸಬೇಕು.

vi) ಈ ಆದೇಶದ ದಿನಾಂಕದಿಂದ ಮೂರು ತಿಂಗಳ ಒಳಗೆ ಸದರಿ ಪ್ರಕ್ರಿಯೆಯನ್ನು ಮುಕ್ತಾಯ ಗೊಳಿಸುವುದು ನಂತರದಲ್ಲಿ, ಯಾವುದೇ ಕಾರಣಕ್ಕೂ ಅಂತಹ ಪ್ರಕರಣಗಳನ್ನು ಪರಿಗಣಿಸತಕ್ಕದ್ದಲ್ಲ.

**ಎ. ಆರ್. ವಿಜಯಾನಂದ ಶರ್ಮ,**
ಸರ್ಕಾರದ ಅಧೀನ ಕಾರ್ಯದರ್ಶಿ,
ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಇಲಾಖೆ

**PR - 2141**

## ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಸಚಿವಾಲಯ

**ವಿಷಯ :** ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಯಲ್ಲಿ ಹೊಸದಾಗಿ ಸೃಜಿಸಿರುವ ವಿಶೇಷ ಕಾರ್ಯದರ್ಶಿ ಹುದ್ದೆಗೆ ಕಾರ್ಯಕಾರಿ ಆದೇಶದ ಮೂಲಕ ನೇಮಕಾತಿ ವಿಧಾನವನ್ನು ನಿಗದಿಪಡಿಸುವ ಕುರಿತು.

**ಉಲ್ಲೇಖ :** 1. ಸರ್ಕಾರಿ ಆದೇಶ ಸಂಖ್ಯೆ : ಸಿಆಸುಇ 200 ಸಅಸೇ 2012, ದಿನಾಂಕ : 09–07–2012.

2. ಅಧಿಕೃತ ಜ್ಞಾಪನ ಸಂಖ್ಯೆ : ಸಿಆಸುಇ 38 ಸೇನಿಇ 1996, ದಿನಾಂಕ : 01–08–1996

**ಪ್ರಸ್ತಾವನೆ :–**

ಮೇಲೆ (1)ರಲ್ಲಿ ಓದಲಾದ ಸರ್ಕಾರಿ ಆದೇಶದಲ್ಲಿ ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಯಲ್ಲಿ ಸಚಿವಾಲಯದ 33 ಇಲಾಖೆಗಳಲ್ಲಿ ಹೊರಡಿಸಿರುವ ಸುಮಾರು 300 ಕ್ಕೂ ಹೆಚ್ಚು ಅಧಿನಿಯಮಗಳನ್ನು ಕ್ರೋಢೀಕರಿಸಿ ತಿದ್ದುಪಡಿಗಳನ್ನು ಸೇರಿಸಿ ಮುದ್ರಿಸಿ ಸಾರ್ವಜನಿಕರಿಗೆ ಲಭ್ಯವಾಗುವಂತೆ ಮಾಡುವ ಕಾರ್ಯವನ್ನು ನಿರ್ವಹಿಸಲು ಒಂದು **ವಿಶೇಷ ಕಾರ್ಯದರ್ಶಿ** (ವೇತನ ಶ್ರೇಣಿ ರೂ. 56,550–79,800) ಹುದ್ದೆಯನ್ನು ಆಪ್ತ ಶಾಖೆಯೊಂದಿಗೆ ಸೃಜಿಸಲಾಗಿದೆ.

ವಿಶೇಷ ಕಾರ್ಯದರ್ಶಿ, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆ, ಹುದ್ದೆಯನ್ನು ವೃಂದ ಮತ್ತು ನೇಮಕಾತಿ ನಿಯಮಗಳಿಗೆ ತಿದ್ದುಪಡಿ ಮಾಡುವ ಮೂಲಕ ವೃಂದ ಮತ್ತು ನೇಮಕಾತಿ ನಿಯಮಗಳಲ್ಲಿ ಅಳವಡಿಸಿ ತುಂಬಲು ಸಾಕಷ್ಟು ಕಾಲಾವಕಾಶ ಬೇಕಾಗುವುದರಿಂದ ಈ ಹುದ್ದೆಯನ್ನು ಕಾರ್ಯಕಾರಿ ಆದೇಶದ ಮೂಲಕ ನೇಮಕಾತಿ ವಿಧಾನವನ್ನು ನಿಗದಿಪಡಿಸಿ ತುಂಬಲು ಅವಕಾಶ ಕಲ್ಪಿಸಲು ಉದ್ದೇಶಿಸಲಾಗಿದೆ. ಈ ಹಿನ್ನೆಲೆಯಲ್ಲಿ ಕರ್ನಾಟಕ ಸರ್ಕಾರ ಸಚಿವಾಲಯ ಸೇವೆಗಳು (ನೇಮಕಾತಿ) ನಿಯಮಗಳು, 1992ಕ್ಕೆ ಸೂಕ್ತ ತಿದ್ದುಪಡಿ ತರುವುದನ್ನು ಕಾಯ್ದಿರಿಸಿ ಮೇಲೆ (2)ರಲ್ಲಿ ಓದಲಾದ ಅಧಿಕೃತ ಜ್ಞಾಪನದಲ್ಲಿನ ಮಾರ್ಗಸೂಚಿಗಳನ್ನು ಅಳವಡಿಸಿಕೊಂಡು ಕಾರ್ಯಕಾರಿ ಆದೇಶ ಹೊರಡಿಸುವ ಮೂಲಕ ಮೇಲ್ಕಂಡ ಹುದ್ದೆಗೆ ನೇಮಕಾತಿ ವಿಧಾನವನ್ನು ಜಾರಿಗೆ ತರಲು ಉದ್ದೇಶಿಸಿ, ಸರ್ಕಾರವು ಈ ಮುಂದಿನಂತೆ ಆದೇಶಿಸಿದೆ.

## ಸರ್ಕಾರದ ಆದೇಶ ಸಂಖ್ಯೆ : ಸಿಆಸುಇ 200 ಸಅಸೇ 2012, ಬೆಂಗಳೂರು, ದಿನಾಂಕ : 10ನೇ ಅಕ್ಟೋಬರ್ 2012

ಪ್ರಸ್ತಾವನೆಯಲ್ಲಿ ವಿವರಿಸಿರುವ ಹಿನ್ನೆಲೆಯಲ್ಲಿ ದಿನಾಂಕ : 09–07–2012ರ ಆದೇಶದನ್ವಯ ಸೃಜಿಸಲಾಗಿರುವ ಕರ್ನಾಟಕ ಸರ್ಕಾರ ಸಚಿವಾಲಯದ ಸೇವೆಗೆ ಸೇರಿವ ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಯ **ವಿಶೇಷ ಕಾರ್ಯದರ್ಶಿ** (ವೇತನ ಶ್ರೇಣಿ ರೂ. 56,550–79,800) ಹುದ್ದೆಗೆ ಕೆಳಕಂಡ ಷರತ್ತುಗಳಿಗೊಳಪಟ್ಟು ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ಈ ಆದೇಶದ ಅನುಬಂಧದಲ್ಲಿ ನಮೂದಿಸಿರುವಂತೆ ನೇಮಕಾತಿ ಕಾರ್ಯವಿಧಾನವನ್ನು ನಿಗದಿಪಡಿಸಲಾಗಿದೆ.

1. ಈ ಕಾರ್ಯಕಾರಿ ಆದೇಶದ ಮೂಲಕ ನಿಗಧಿಪಡಿಸಿದ ನೇಮಕಾತಿ ವಿಧಾನವು ಸದರಿ ಕಾರ್ಯಕಾರಿ ಆದೇಶವನ್ನು ಹೊರಡಿಸಿದ ದಿನಾಂಕದಿಂದ ಆರು ತಿಂಗಳ ಕಾಲ ಮಾತ್ರ ಜಾರಿಯಲ್ಲಿರುತ್ತದೆ.
2. ಆರು ತಿಂಗಳ ಒಳಗಾಗಿ ಈ ನೇಮಕಾತಿ ಕಾರ್ಯ ವಿಧಾನವನ್ನು ಕರ್ನಾಟಕ ಸರ್ಕಾರದ ಸಚಿವಾಲಯ ಸೇವೆಗಳು (ನೇಮಕಾತಿ) ನಿಯಮಗಳಿಗೆ ತಿದ್ದುಪಡಿ ಮಾಡಿ ಅಳವಡಿಸತಕ್ಕದ್ದು.
3. ಆರು ತಿಂಗಳ ನಂತರ ಈ ಕಾರ್ಯಕಾರಿ ಆದೇಶವು ತನ್ನಿಂದ ತಾನೇ ರದ್ದಾಗುತ್ತದೆ.

ಈ ಆದೇಶವನ್ನು ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವಾ ನಿಯಮಗಳು) ದಿನಾಂಕ ; 28–09–2012ರ ಟಿಪ್ಪಣೆ ಸಂಖ್ಯೆ : ಸಿಆಸುಇ 123 ಸೇನಿಡಿ 2012ರಲ್ಲಿ ನೀಡಿರುವ ಸಹಮತಿಯನ್ವಯ ಹೊರಡಿಸಲಾಗಿದೆ.

**ಅನುಬಂಧ**

| ಹುದ್ದೆಯ ಪದನಾಮ ಮತ್ತು ವೇತನ ಶ್ರೇಣಿ | ಹುದ್ದೆಗಳ ಸಂಖ್ಯೆ | ನೇಮಕಾತಿ ವಿಧಾನ | ಕನಿಷ್ಠ ಅರ್ಹತೆ |
|---|---|---|---|
| ವಿಶೇಷ ಕಾರ್ಯದರ್ಶಿ, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆ | 1 | ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಯ ಅಪರ ಕಾರ್ಯದರ್ಶಿ ವೃಂದದಿಂದ ಆಯ್ಕೆ ಮೂಲಕ ಬಡ್ತಿ | ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಯಲ್ಲಿನ ಅಪರ ಕಾರ್ಯದರ್ಶಿ ವೃಂದದಲ್ಲಿ ಕನಿಷ್ಠ 5 ವರ್ಷಗಳ ಸೇವೆ ಸಲ್ಲಿಸಿರಬೇಕು |

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ
**ಹೆಚ್. ಕೆ. ಲಕ್ಷ್ಮೀನಾರಾಯಣ ರಾವ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3)

**PR - 2142**

## ಒಳಾಡಳಿತ ಸಚಿವಾಲಯ

## ತಿದ್ದೋಲೆ

**ಸಂಖ್ಯೆ : ಹೆಚ್‌ಡಿ 11 ಪಿಸಿಇ 2012, ಬೆಂಗಳೂರು, ದಿನಾಂಕ : 29ನೇ ಸೆಪ್ಟೆಂಬರ್, 2012**

**ವಿಷಯ :** ದಿನಾಂಕ : 02–03–2012ರಂದು ಬೆಂಗಳೂರು ನಗರದ ಸಿವಿಲ್ ನ್ಯಾಯಾಲಯದ ಆವರಣದಲ್ಲಿ ವಕೀಲರು, ಮಾಧ್ಯಮ ಪ್ರತಿನಿಧಿಗಳು ಮತ್ತು ಪೊಲೀಸ್ ನಡುವೆ ನಡೆದ ಘಟನೆಯ ಹಿನ್ನೆಲೆಯ್ಲುಲಿ ರಚಿಸಲಾದ ವಿಚಾರಣಾ ಆಯೋಗದ ಮುಂದೆ ಪೊಲೀಸರ ಪರವಾಗಿ ವಾದ ಮಂಡಿಸಲು ಶ್ರೀ ತಿಮ್ಮರಾಯಪ್ಪ, ಹಿರಿಯ ವಕೀಲರು, ಶ್ರೀ ಹೆಚ್. ವಿ. ರಮೇಶ್, ವಕೀಲರು ಇವರುಗಳೀಗೆ ಸಂಭಾವನೆ ಪಾವತಿಸುವ ಬಗ್ಗೆ.

ಸರ್ಕಾರದ ಆದೇಶ ಸಂಖ್ಯೆ : ಹೆಚ್ ಡಿ 11 ಪಿಸಿಇ 2012, ಬೆಂಗಳೂರು ದಿನಾಂಕ : 13–08–2012ರ ಆದೇಶದಲ್ಲಿನ 2ನೇ ಕಂಡಿಕೆ **"ಪ್ರಸ್ತಾಪಿತ ಸಂಭಾವನೆಯನ್ನು ಲೆಕ್ಕ ಶೀರ್ಷಿಕೆ 2055–00–108–0–01–05 ರಡಿಯಲ್ಲಿ ಭರಿಸತಕ್ಕದ್ದು"** ಎಂಬುದರ ಬದಲಾಗಿ **"ಪ್ರಸ್ತಾಪಿತ ಸಂಭಾವನೆಯನ್ನು ಲೆಕ್ಕ ಶೀರ್ಷಿಕೆ 2055–00–108–0–01 015ರಡಿಯಲ್ಲಿ ಭರಿಸತಕ್ಕದ್ದು"** ಎಂದು ಓದಿಕೊಳ್ಳತಕ್ಕದ್ದು. ಸದರಿ ಆದೇಶದಲ್ಲಿ ಇನ್ನಾವುದೇ ಬದಲಾವಣೆಗಳು ಇರುವುದಿಲ್ಲ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,
**ಪ್ರಕಾಶ ವೈ. ಕೆ.**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಕಾನೂನು ಮತ್ತು ಸುವ್ಯವಸ್ಥೆ).

**PR - 2143**

## ಒಳಾಡಳಿತ ಸಚಿವಾಲಯ

**ವಿಷಯ :** ಕೇಂದ್ರಿಯ ಗುಪ್ತಚಾರ ವಿಭಾಗ, ಭಾರತ ಸರ್ಕಾರದ ಗೃಹ ಮಂತ್ರಾಲಯ, ನಂ. 25, ಇನ್‌ಫೆಂಟ್ರಿ ರಸ್ತೆ ಮತ್ತು ಕಾವೇರಿ ಭವನ, ಬೆಂಗಳೂರು ಇಲ್ಲಿಗೆ ಒದಗಿಸಿರುವ ಸಶಸ್ತ್ರ ರಕ್ಷಣಾ ಪಡೆಯನ್ನು ಮುಂದುವರೆಸುವ ಬಗ್ಗೆ.

**ಓದಲಾಗಿದೆ :** 1) ಸರ್ಕಾರದ ಆದೇಶ ಸಂಖ್ಯೆ : ಒಇ 122 ಪಿಓಪಿ 2011, ದಿನಾಂಕ : 04–07–2011.

2) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು ರವರ ಪತ್ರ ಸಂಖ್ಯೆ : ಆರ್.ಎಲ್.ಎನ್. (3)95/1991–92, ದಿನಾಂಕ : 29–02–2012 ಹಾಗೂ 07–07–2012.

**ಪ್ರಸ್ತಾವನೆ :**

ಮೇಲೆ ಓದಲಾದ (1)ರ ಕೇಂದ್ರಿಯ ಗುಪ್ತಚಾರ ವಿಭಾಗ, ಭಾರತ ಸರ್ಕಾರದ ಗೃಹ ಮಂತ್ರಾಲಯ, ನಂ. 25, ಇನ್‌ಫೆಂಟ್ರಿ ರಸ್ತೆ, ಬೆಂಗಳೂರು ಇಲ್ಲಿಗೆ ಎಹೆಚ್‌ಸಿ–1 ಮತ್ತು ಎಪಿಸಿ–4 ಹಾಗೂ ಕಾವೇರಿ ಭವನ, ಬೆಂಗಳೂರು ಇಲ್ಲಿಗೆ ಒದಗಿಸಿರುವ ಸಶಸ್ತ್ರ ರಕ್ಷಣಾ ಪಡೆಯ ಸಿಬ್ಬಂದಿಗಳಾದ ಎಹೆಚ್‌ಸಿ–1 ಎಪಿಸಿ–4 ಹುದ್ದೆಗಳನ್ನು ದಿನಾಂಕ : 01–05–2011 ರಿಂದ ಒಂದು ವರ್ಷದ ಅವಧಿಗೆ ತಾತ್ಕಾಲಿಕವಾಗಿ ಮುಂದುವರೆಸಿದೆ.

ಮೇಲೆ ಓದಲಾದ (2)ರ ಪತ್ರದಲ್ಲಿ ಕೇಂದ್ರಿಯ ಗುಪ್ತಚಾರ ವಿಭಾಗ, ಭಾರತ ಸರ್ಕಾರದ ಗೃಹ ಮಂತ್ರಾಲಯ, ನಂ. 25, ಇನ್‌ಫೆಂಟ್ರಿ ರಸ್ತೆ, ಬೆಂಗಳೂರು ಇಲ್ಲಿಗೆ ಎಹೆಚ್‌ಸಿ–**1 ಮತ್ತು** ಎಪಿಸಿ–**4** ಹಾಗೂ ಕಾವೇರಿ ಭವನ, ಬೆಂಗಳೂರು ಇಲ್ಲಿಗೆ ಎಹೆಚ್‌ಸಿ–1 ಮತ್ತು ಎಪಿಸಿ–4 ಹುದ್ದೆಗಳ ಅವಧಿಯು ದಿನಾಂಖ ; 30–04–2012ಕ್ಕೆ ಮುಕ್ತಾಯವಾಗುವುದರಿಂದ ಸದರಿ ಹುದ್ದೆಗಳ ಅವಶ್ಯಕತೆಯಿರುವುದರಿಂದ ದಿನಾಂಕ : 01–05–2012 ರಿಂದ 1 ವರ್ಷದ ಅವಧಿಗೆ ಮುಂದುವರೆಸುವಂತೆ ಕೋರಿರುತ್ತಾರೆ.

ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರ ಪ್ರಸ್ತಾವನೆಯನ್ನು ಪರಿಶೀಲಿಸಿ ಈ ಕಳಕಂಡಂತೆ ಆದೇಶ ಹೊರಡಿಸಲಾಗಿದೆ.

**ಸರ್ಕಾರದ ಆದೇಶ ಸಂಖ್ಯೆ : ಹೆಚ್‌ಡಿ 75 ಪಿಓಪಿ 2012, ಬೆಂಗಳೂರು, ದಿನಾಂಕ : 17ನೇ ಆಗಸ್ಟ್, 2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಹಿನ್ನೆಲೆಯಲ್ಲಿ, ಕೇಂದ್ರಿಯ ಗುಪ್ತಚಾರ ವಿಭಾಗ, ಭಾರತ ಸರ್ಕಾರದ ಗೃಹ ಮಂತ್ರಾಲಯ, ನಂ. 25, ಇನ್‌ಫೆಂಟ್ರಿ ರಸ್ತೆ, ಬೆಂಗಳೂರು ಹಾಗೂ ಕಾವೇರಿ ಭವನ, ಬೆಂಗಳೂರು ಇಲ್ಲಿಗೆ ಒಟ್ಟು ಎಹೆಚ್‌ಸಿ–2 ಮತ್ತು ಎಪಿಸಿ–8 ಹುದ್ದೆಗಳನ್ನು ದಿನಾಂಕ : 01–05–2012ರಿಂದ 1 ವರ್ಷದ ಅವಧಿಗೆ ಅಥವಾ ಕರ್ನಾಟಕ ರಾಜ್ಯ ಇಂಡಸ್ಟ್ರಿಯಲ್ ಸೆಕ್ಯೂರಿಟಿ ಫೋರ್ಸ್‌ಗೆ ಸೃಜಿಸಲಾದ ಹುದ್ದೆಗಳ ಪೈಕಿ ಸದರಿ ಹುದ್ದೆಗಳನ್ನು ನಿಯೋಜಿಸುವವರೆಗೆ ಇವುಗಳಲ್ಲಿ ಯಾವುದು ಮೊದಲೋ ಅಲ್ಲಿಯವರೆಗೆ ಹುದ್ದೆಗಳನ್ನು ತಾತ್ಕಾಲಿಕವಾಗಿ ಮುಂದುವರೆಸಿ ಸರ್ಕಾರದ ಮಂಜೂರಾತಿ ನೀಡಿದೆ.

ಈ ಆದೇಶವನ್ನು ಆಂತರಿಕ ಆರ್ಥಿಕ ಸಲಹೆಗಾರರ ಟಿಪ್ಪಣಿ ಸಂಖ್ಯೆ : ಒಸಾಇ 39021 ಆಂಆಸ 2012, ದಿನಾಂಕ : 30–07–2012ರಲ್ಲಿ ನೀಡಿದ ಸಹಮತಿ ಹಾಗೂ ಸರ್ಕಾರದ ಆದೇಶ ಸಂಖ್ಯೆ : ಎಫ್‌ಡಿ 04 ಟಿಎಫ್‌ಪಿ 2012, ದಿನಾಂಕ : 27–04–2012ರಲ್ಲಿ ಸರ್ಕಾರದ ಪ್ರಧಾನ ಕಾರ್ಯದರ್ಶಿ/ಕಾರ್ಯದರ್ಶಿಯವರಿಗೆ ಪ್ರತ್ಯಾಯೋಜಿಸಿರುವ ಅಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಹೆಚ್. ಆರ್. ಪುಟ್ಟೇಗೌಡ,**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಪೊಲೀಸ್ ವೆಚ್ಚ).

**PR - 2144**

## ಒಳಾಡಳಿತ ಸಚಿವಾಲಯ

**ವಿಷಯ :** ಪೊಲೀಸ್ ಇನ್ಸ್‌ಪೆಕ್ಟರ್ (ಸಿವಿಲ್) ಹುದ್ದೆಯಿಂದ ಡೆಪ್ಯೂಟಿ ಸೂಪರಿಂಟೆಂಡೆಂಟ್ ಆಫ್ ಪೊಲೀಸ್ (ಸಿವಿಲ್) ಹುದ್ದೆಗೆ ಮೇಲ್ದರ್ಜೆಗೇರಿಸಲಾದ ಹುದ್ದೆಗಳನ್ನು ಮುಂದುವರೆಸುವ ಬಗ್ಗೆ.

**ಓದಲಾಗಿದೆ :** 1) ಸರ್ಕಾರದ ಆದೇಶ ಸಂಖ್ಯೆ : 72 ಪಿಓಪಿ 2011, ದಿನಾಂಕ : 08–04–2011.

2) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು ರವರ ಪತ್ರ ಸಂಖ್ಯೆ : ಆರ್.ಎಲ್.ಎನ್.(2)/5/2006–07, ದಿನಾಂಕ : 19–04–2012.

**ಪ್ರಸ್ತಾವನೆ :**

ಮೇಲೆ ಓದಲಾದ (1)ರ ಆದೇಶದಲ್ಲಿ, ಡಿ.ವೈ.ಎಸ್.ಪಿ (ಸಿವಿಲ್) 50 ಹುದ್ದೆಗಳನ್ನು (ಸಿ.ಓ.ಡಿ. ಘಟಕದ 30, ರಾಜ್ಯ ಗುಪ್ತವಾರ್ತೆ ಘಟಕದ 20 ಪಿ.ಐ. ಸಿವಿಲ್ ಮೇಲ್ದರ್ಜೆಗೇರಿಸಿದ) ದಿನಾಂಕ : 18–04–2011 ರಿಂದ ಒಂದು ವರ್ಷದ ಅವಧಿಗೆ ತಾತ್ಕಾಲಿಕವಾಗಿ ಮುಂದುವರೆಸಿದೆ.

ಮೇಲೆ ಓದಲಾದ (2)ರ ಪತ್ರದಲ್ಲಿ ಸದರಿ ಹುದ್ದೆಗಳ ಅವಧಿಯು ದಿನಾಂಕ ; 17–04–2012ಕ್ಕೆ ಮುಕ್ತಾಯವಾಗುವುದರಿಂದ ಸದರಿ ಹುದ್ದೆಗಳ ಅವಶ್ಯಕತೆಯಿರುವುದರಿಂದ ದಿನಾಂಕ : 18–04–2012 ರಿಂದ 1 ವರ್ಷದ ಅವಧಿಗೆ ಮುಂದುವರೆಸುವಂತೆ ಕೋರಿರುತ್ತಾರೆ.

ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರ ಪ್ರಸ್ತಾವನೆಯನ್ನು ಪರಿಶೀಲಿಸಿ ಈ ಕೆಳಕಂಡಂತೆ ಆದೇಶ ಹೊರಡಿಸಲಾಗಿದೆ.

**ಸರ್ಕಾರದ ಆದೇಶ ಸಂಖ್ಯೆ : ಹೆಚ್‌ಡಿ 134 ಪಿಓಪಿ 2012, ಬೆಂಗಳೂರು, ದಿನಾಂಕ : 01ನೇ ಆಗಸ್ಟ್, 2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ, ಡಿ.ವೈ.ಎಸ್.ಪಿ. (ಸಿವಿಲ್) 50 ಹುದ್ದೆಗಳನ್ನು (ಸಿ.ಓ.ಡಿ. ಘಟಕದ 30, ರಾಜ್ಯ ಗುಪ್ತವಾರ್ತೆ ಘಟಕದ 20 ಪಿ.ಐ. ಸಿವಿಲ್ ಮೇಲ್ದರ್ಜೆಗೇರಿಸಿದ) ದಿನಾಂಕ : 18–04–2012ರಿಂದ 1 (ಒಂದು) ವರ್ಷದ ಅವಧಿಗೆ ತಾತ್ಕಾಲಿಕವಾಗಿ ಮುಂದುವರೆಸಿ ಸರ್ಕಾರದ ಮಂಜೂರಾತಿ ನೀಡಿದೆ.

ಈ ಆದೇಶವನ್ನು ಆಂತರಿಕ ಆರ್ಥಿಕ ಸಲಹೆಗಾರರ ಟಿಪ್ಪಣಿ ಸಂಖ್ಯೆ : ಒಸಾಇ 37191 ಆಂಆಸ 2012, ದಿನಾಂಕ : 23–07–2012ರಲ್ಲಿ ನೀಡಿದ ಸಹಮತಿ ಹಾಗೂ ಸರ್ಕಾರದ ಆದೇಶ ಸಂಖ್ಯೆ : ಎಫ್‌ಡಿ 01 ಟಿಎಫ್‌ಪಿ 2008, ದಿನಾಂಕ : 16–05–2008ರಲ್ಲಿ ಸರ್ಕಾರದ ಪ್ರಧಾನ ಕಾರ್ಯದರ್ಶಿ/ಕಾರ್ಯದರ್ಶಿಯವರಿಗೆ ಪ್ರತ್ಯಾಯೋಜಿಸಿರುವ ಅಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಹೆಚ್. ಆರ್. ಪುಟ್ಟೇಗೌಡ,**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಪೊಲೀಸ್ ವೆಚ್ಚ).

**PR - 2145**

## ಒಳಾಡಳಿತ ಸಚಿವಾಲಯ

**ವಿಷಯ :** 9ನೇ ಪಡೆ, ಕೆ.ಎಸ್.ಆರ್.ಪಿ. ಬೆಂಗಳೂರು, ಕೂಡ್ಲು ಘಟಕಕ್ಕೆ ಕಾವೇರಿ ನೀರು ಸರಬರಾಜು ಮಾಡುವ ಯೋಜನೆಗೆ ಅಗತ್ಯವಿರುವ ರೂ. 96,15,000/–ಗಳನ್ನು ಬಿಡುಗಡೆ ಮಾಡುವ ಬಗ್ಗೆ.

**ಓದಲಾಗಿದೆ :** ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರವರ ಪತ್ರ ಸಂಖ್ಯೆ : ಬಿ1ಸಿ/89/2011–12, ದಿನಾಂಕ : 16–06–2012

**ಪ್ರಸ್ತಾವನೆ :**

ಮೇಲೆ ಓದಲಾದ ದಿನಾಂಕ : 16–06–2012ರ ಪತ್ರದಲ್ಲಿ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರುರವರು ಸರ್ಕಾರಕ್ಕೆ ಪ್ರಸ್ತಾವನೆ ಸಲ್ಲಿಸಿ, 9ನೇ ಪಡೆ, ಕೆ.ಎಸ್.ಆರ್.ಪಿ. ಬೆಂಗಳೂರು, ಕೂಡ್ಲು ಘಟಕಕ್ಕೆ ಕಾವೇರಿ ನೀರು ಸರಬರಾಜು ಮಾಡುವ ಯೋಜನೆಗೆ

ಸಂಬಂಧಿಸಿದಂತೆ 2009–10ನೇ ಸಾಲಿನ 12ನೇ ಹಣಕಾಸು ಯೋಜನೆಯಡಿ ರೂ. 1.30 ಕೋಟಿ ಅನುದಾನ ನೀಡಲಾಗಿದೆ. ಬೆಂಗಳೂರು ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿರವರು ನಿಗದಿಪಡಿಸಿದ ಅಂದಾಜು ಪಟ್ಟಿ ಪ್ರಕಾರ ಇನ್ನು ರೂ. 1,34,14,037/–ಗಳನ್ನು ಠೇವಣಿ ಇರಿಸಿದಲ್ಲಿ ಕಾಮಗಾರಿ ಪ್ರಾರಂಭಿಸುವುದಾಗಿ ತಿಳಿಸಿರುವುದರಿಂದ ಸದರಿ ಕಾಮಗಾರಿಗೆ ಈಗಾಗಲೇ ಸರ್ಕಾರವು ಬಿಡುಗಡೆ ಮಾಡಿರುವ ಅನುದಾನವು ಸೇರಿದಂತೆ ಒಟ್ಟು ರೂ. 2,64,14,000/–ಗಳನ್ನು ಬೆಂಗಳೂರು ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿಯಲ್ಲಿ ಠೇವಣಿ ಇಡಲಾಗಿದೆ. ಆದರೆ, ಪೈಪ್‌ಲೈನ್ ಹಾದು ಹೋಗುವ ಮಾರ್ಗದಲ್ಲಿ ಖಾಸಗಿ ವ್ಯಕ್ತಿಗಳು ಅವರ ನಿವೇಶನಗಳ/ಜಮೀನಿಗಳು ಅಡ್ಡಿ ಬಂದಿರುವುದರಿಂದ ಖಾಸಗಿ ವ್ಯಕ್ತಿಗಳು ಅವರ ನಿವೇಶನ/ಜಮೀನುಗಳಲ್ಲಿ ಪೈಪ್‌ಲೈನ್ ಹಾಕಲು ಅವಕಾಶ ನೀಡುತ್ತಿಲ್ಲವಾದ್ದರಿಂದ ಪೈಪ್‌ಲೈನ್ ದಾರಿ ಬದಲಿಸಬೇಕಾಗಿ ಬಂದಿದ್ದು, ಇದಕ್ಕೆ ಹೆಚ್ಚುವರಿಯಾಗಿ ರೂ. 76,50,000/– ಬೇಕಾಗಿರುತ್ತದೆ. ಅಲ್ಲದೆ ಪರಿಷ್ಕೃತ ಅಂದಾಜುಪಟ್ಟಿ ಪ್ರಕಾರ ಪೈಪ್‌ಲೈನ್‌ಗೆ ರೂ. 1,96,50,000 ಆಗಲಿದ್ದು, ಒಟ್ಟು ಅಂದಾಜು 3,40,64,547/–ಗಳ ಆಗಿರುತ್ತದೆ. ಮಾರುಕಟ್ಟೆಯಲ್ಲಿ ಕಾಮಗಾರಿಯ ಎಲ್ಲಾ ಸಾಮಗ್ರಿಗಳ ವೆಚ್ಚ ಮತ್ತು ಕಾಮಗಾರಿಯ ಮಜೂರಿ ದಿನೇ ದಿನೇ ಶೇಕಡ 10 ರಿಂದ 15 ರಷ್ಟು ಹೆಚ್ಚು ತುಟ್ಟಿಯಾಗುವ ಸಾಧ್ಯತೆ ಇರುವ ಕಾರಣ ಸದರಿ ಕಾಮಗಾರಿ ಅಂದಾಜು ಪಟ್ಟಿಗೆ ಕೂಡಲೇ ಶೇಕಡ 10ರಷ್ಟು ಹೆಚ್ಚಿನ ಮೊತ್ತ ಅಂದರೆ ರೂ. 19.65 ಲಕ್ಷಗಳು ಮತ್ತು ಬಾಕಿ ಮೊತ್ತ 76.50 ಲಕ್ಷ ಸೇರಿ ಒಟ್ಟಾರೆ ರೂ. 96,15,000/–ಗಳ ಅನುದಾನವನ್ನು ಬೆಂಗಳೂರು ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿರವರಲ್ಲಿ ಠೇವಣಿ ಇರಿಸಲು 2012–13ನೇ ಸಾಲಿನ ಲೆಕ್ಕ ಶೀರ್ಷಿಕೆ 2055–00–104–0–01–059 ಇತರೆ ವೆಚ್ಚ ಇದರಡಿಯಲ್ಲಿ ಕಮಾಂಡೆಂಟ್ 9ನೇ ಪಡೆ ಕೆ.ಎಸ್.ಆರ್.ಪಿ. ಬೆಂಗಳೂರು ರವರಿಗೆ ಬಿಡುಗಡೆ ಮಾಡುವಂತೆ ಕೋರಿರುತ್ತಾರೆ.

ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರವರ ಪ್ರಸ್ತಾವನೆಯನ್ನು ಪರಿಶೀಲಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಹೆಚ್‌ಡಿ 67 ಪಿಬಿಎಲ್ 2012, ಬೆಂಗಳೂರು, ದಿನಾಂಕ : 27ನೇ ಜುಲೈ, 2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ, 9ನೇ ಪಡೆ, ಕೆ.ಎಸ್.ಆರ್.ಪಿ. ಬೆಂಗಳೂರು, ಕೂಡ್ಲು ಘಟಕಕ್ಕೆ ಕಾವೇರಿ ನೀರು ಸರಬರಾಜು ಮಾಡುವ ಯೋಜನೆಗೆ ಪೈಪ್‌ಲೈನ್ ಹಾದು ಹೋಗುವ ಮಾರ್ಗದಲ್ಲಿ ಖಾಸಗಿ ವ್ಯಕ್ತಿಗಳು ಅವರ ನಿವೇಶನಗಳ/ಜಮೀನುಗಳು ಅಡ್ಡಿ ಬಂದಿರುವುದರಿಂದ ಪೈಪ್‌ಲೈನ್ ದಾರಿ ಬದಲಿಸಿ ಅಳವಡಿಸಲು ತಗಲುವ ವೆಚ್ಚ ರೂ. 96,15,000/–ಗಳನ್ನು (ತೊಂಬತ್ತಾರು ಲಕ್ಷದ ಹದಿನೈದು ಸಾವಿರ ರೂಪಾಯಿಗಳು ಮಾತ್ರ) ಬೆಂಗಳೂರು ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿರವರಲ್ಲಿ ಠೇವಣಿ ಇರಿಸಲು ಕಮಾಂಡೆಂಟ್ 9ನೇ ಪಡೆ ಕೆ.ಎಸ್.ಆರ್.ಪಿ. ಬೆಂಗಳೂರು ರವರಿಗೆ ಬಿಡುಗಡೆ ಮಾಡಲು ಸರ್ಕಾರದ ಮಂಜೂರಾತಿಯನ್ನು ನೀಡಲಾಗಿದೆ.

ಈ ವೆಚ್ಚವನ್ನು 2012–13ನೇ ಸಾಲಿನ ಲೆಕ್ಕ ಶೀರ್ಷಿಕೆ 2055–00–104–0–01–059 ಇತರೆ ವೆಚ್ಚಗಳು (ಯೋಜನೇತರ) ಅಡಿಯಲ್ಲಿ ಲಭ್ಯವಿರುವ ಅನುದಾನದಿಂದ ಭರಿಸತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ : ಆಇ 255 ವೆಚ್ಚ 11/2012 ದಿನಾಂಕ : 20–07–2012 ನೀಡಿರುವ ಸಹಮತಿ ಹಾಗೂ ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಆಇ:01:ಟಿಎಫ್‌ಪಿ:2011 ದಿನಾಂಕ : 28–09–2011ರಲ್ಲಿ ಇಲಾಖಾ ಕಾರ್ಯದರ್ಶಿಗಳಿಗೆ ಪ್ರತ್ಯಾಯೋಜಿಸಲಾದ ಆರ್ಥಿಕ ಅಧಿಕಾರದನ್ವಯ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,
**ಹೆಚ್. ಆರ್. ಪುಟ್ಟೇಗೌಡ,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ವೆಚ್ಚ).

**PR - 2146**

## ಒಳಾಡಳಿತ ಸಚಿವಾಲಯ

**ವಿಷಯ :** ನ್ಯಾಯಮೂರ್ತಿ ಶ್ರೀ ಆರ್.ಜಿ. ವೈದ್ಯನಾಥ ವಿಚಾರಣಾ ಆಯೋಗಕ್ಕೆ ಹಣ ಬಿಡುಗಡೆ ಮಾಡುವ ಬಗ್ಗೆ.

**ಓದಲಾಗಿದೆ :** 1) ಅಧಿಸೂಚನೆ ಸಂಖ್ಯೆ : ಹೆಚ್‌ಡಿ 4 ಪಿಸಿಇ 2012, ದಿನಾಂಕ : 09–03–2012.

2) ಸರ್ಕಾರದ ಆದೇಶ ಸಂಖ್ಯೆ : ಹೆಚ್‌ಡಿ 4 ಪಿಸಿಇ 2012 (ಭಾಗ–4) ದಿನಾಂಕ : 09–07–2012.

3) ಕಾರ್ಯದರ್ಶಿ, ನ್ಯಾಯಮೂರ್ತಿ ಶ್ರೀ ಆರ್.ಜಿ. ವೈದ್ಯನಾಥ ವಿಚಾರಣಾ ಆಯೋಗರವರ ಪತ್ರ ಸಂಖ್ಯೆ : ಆರ್‌ಜಿವಿಸಿ ನಂ. 138/2012, ದಿನಾಂಕ : 18–09–2012

**ಪ್ರಸ್ತಾವನೆ :**

ಮೇಲೆ (1)ರಲ್ಲಿ ಓದಲಾದ ಅಧಿಸೂಚನೆ ದಿನಾಂಕ : 02–03–2012ರಂದು ಸಿಟಿ ಸಿವಿಲ್ ನ್ಯಾಯಾಲಯ, ಬೆಂಗಳೂರು ಇಲ್ಲಿ ವಕೀಲರು, ಮಾಧ್ಯಮ ಪ್ರತಿ ನಿಧಿಗಳು ಮತ್ತು ಪೊಲೀಸರ ನಡುವೆ ನಡೆದ ಘರ್ಷಣೆಯ ಕುರಿತು ಸತ್ಯಾ ಸತ್ಯತೆಯನ್ನು ತಿಳಿದುಕೊಳ್ಳಲು ನ್ಯಾಯಮೂರ್ತಿ ಶ್ರೀ ಆರ್.ಜಿ. ವೈದ್ಯನಾಥ, ನಿವೃತ್ತ ನ್ಯಾಯಾಧೀಶರು ಇವರ ನೇತೃತ್ವದಲ್ಲಿ ಏಕ ಸದಸ್ಯ ವಿಚಾರಣಾ ಆಯೋಗವನ್ನು ರಚಿಸಲಾಗಿದೆ. ಮೇಲೆ (2)ರಲ್ಲಿ ಓದಲಾದ ಸರ್ಕಾರಿ ಆದೇಶದಲ್ಲಿ ನ್ಯಾಯಮೂರ್ತಿ ಶ್ರೀ ಆರ್.ಜಿ. ವೈದ್ಯನಾಥ ವಿಚಾರಣಾ ಆಯೋಗದವರು ಸದರಿ ಆಯೋಗದ ಸಹಾಯಕ ಸಿಬ್ಬಂದಿಯ ವೇತನ, ಪ್ರಾಸಂಗಿಕ ಖರ್ಚು–ವೆಚ್ಚ ಹಾಗೂ ಲೇಖನ ಸಾಮಗ್ರಿಗಳು ಮತ್ತು ಇತರೆ ಸಾಮಗ್ರಿಗಳನ್ನು ಖರೀದಿಸಲು ಅನುಕೂಲವಾಗುವಂತೆ ₹ 15,00,000/– (ರೂಪಾಯಿ ಹದಿನೈದು ಲಕ್ಷಗಳು ಮಾತ್ರ)ಗಳನ್ನು ಬಿಡುಗಡೆ ಮಾಡಲಾಗಿತ್ತು. ಮೇಲೆ (3)ರಲ್ಲಿ ಓದಲಾದ ಪತ್ರದಲ್ಲಿ ಕಾರ್ಯದರ್ಶಿ, ನ್ಯಾಯಮೂರ್ತಿ, ಆರ್. ಜಿ. ವೈದ್ಯನಾಥ ವಿಚಾರಣಾ ಆಯೋಗ ಅವರು ಆಯೋಗವು ಡಿಸೆಂಬರ್–2012ರವರೆಗೆ ಸಾಕ್ಷಿದಾರರಿಗೆ ಬಾಟ, ಪ್ರಯಾಣ ಭತ್ಯೆ ಮತ್ತು ನ್ಯಾಯಾಧೀಶರ, ಕಾರ್ಯದರ್ಶಿ ಮತ್ತು ಸಿಬ್ಬಂದಿರವರ ಸಂಬಳ, ವಕೀಲರ ಶುಲ್ಕ, ಲಾ ಬುಕ್‌ಗಳನ್ನು ಖರೀದಿಸಲು, ಕಂಪ್ಯೂಟರ್‌ಗಳ ರಿಪೇರಿ, ಇತರೆ ಪ್ರಾಸಂಗಿಕ ಖರ್ಚು–ವೆಚ್ಚಗಳಿಗಾಗಿ ಹೆಚ್ಚುವರಿ ₹ 30,00,000/– (ರೂಪಾಯಿ ಮೂವತ್ತು ಲಕ್ಷಗಳು ಮಾತ್ರ)ಗಳನ್ನು ಬಿಡುಗಡೆ ಮಾಡುವಂತೆ ಸರ್ಕಾರವನ್ನು ಕೋರಿರುತ್ತಾರೆ. ಪ್ರಸ್ತಾವನೆಯನ್ನು ಸರ್ಕಾರವು ಕೂಲಂಕುಷವಾಗಿ ಪರಿಶೀಲಿಸಿದೆ. ಆದ್ದರಿಂದ ಈ ಆದೇಶ ಹೊರಡಿಸಲಾಗಿದೆ.

**ಸರ್ಕಾರದ ಆದೇಶ ಸಂಖ್ಯೆ : ಹೆಚ್‌ಡಿ 4 ಪಿಸಿಇ 2012 (ಭಾಗ–4) ಬೆಂಗಳೂರು, ದಿನಾಂಕ : 04ನೇ ಅಕ್ಟೋಬರ್, 2012**

ನ್ಯಾಯಮೂರ್ತಿ ಶ್ರೀ ಆರ್. ಜಿ. ವೈದ್ಯನಾಥ, ವಿಚಾರಣಾ ಆಯೋಗಕ್ಕೆ ಸಹಾಯಕ ಸಿಬ್ಬಂದಿಯ ವೇತನ ಪ್ರಾಸಂಗಿಕ ಖರ್ಚು–ವೆಚ್ಚ ಹಾಗೂ ಲೇಖನ ಸಾಮಗ್ರಿಗಳು ಮತ್ತು ಇತರೆ ಸಾಮಗ್ರಿಗಳನ್ನು ಖರೀದಿಸಲು ಅನುಕೂಲವಾಗುವಂತೆ 2012–2013ನೇ ಸಾಲಿಗೆ ₹ 20,00,000/– (ರೂಪಾಯಿ ಇಪ್ಪತ್ತು ಲಕ್ಷಗಳು ಮಾತ್ರ)ಗಳನ್ನು ಲೆಕ್ಕ ಶೀರ್ಷಿಕೆ "2070–00–105–0–02–059 ಇತರ ವಿಚಾರಣಾ ಆಯೋಗ" ಅಡಿಯಲ್ಲಿ ಭರಿಸುವಂತೆ ಹೆಚ್ಚುವರಿ ಹಣವನ್ನು ಸರ್ಕಾರವು ಬಿಡುಗಡೆ ಮಾಡಿದೆ.

ಸದರಿ ಆಯೋಗದ ಕಾರ್ಯದರ್ಶಿಯವರು ಹಣವನ್ನು ಹಿಂತೆಗೆಯುವ ಮತ್ತು ವಿತರಿಸುವ ಅಧಿಕಾರಿಯಾಗಿ ಕರ್ತವ್ಯ ನಿರ್ವಹಿಸುವರು.

ಸರ್ಕಾರದ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 96 ದಿನಾಂಕ : 10–07–1996ರಲ್ಲಿ ಸರ್ಕಾರದ ಪ್ರಧಾನ ಕಾರ್ಯದರ್ಶಿಗಳಿಗೆ ನೀಡಿರುವ ಅಧಿಕಾರ ಪ್ರತ್ಯಾಯೋಜನೆ ರೀತ್ಯಾ ಈ ಆದೇಶವನ್ನು ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,
**ಪ್ರಕಾಶ ವೈ. ಕೆ.**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಕಾನೂನು ಮತ್ತು ಸುವ್ಯವಸ್ಥೆ).

**PR - 2147**

## HOME SECRETARIAT

**CORRIGENDUM**

**Sub :** Sagar Kavach Exercise

**Read :** Govt. Order No. HD 173 SST 2011(P2), Bangalore dated : 04-06-2012

**GOVERNMENT ORDER NO. HD 173 SST 2011(P2) BANGALORE, DATED 04-10-2012**

In the Government Order referred above, in Para 2, line 8, the words "It would be more appropriate to hold Sagar Kavach briefing and de-briefing meetings under the Chairmanship of the concerned Deputy Commissioner", shall be deleted.

In the Order portion para 1, line 2, the sentence, "All briefing and de-briefing meetings of Sagar Kavach Exercise shall be made under his/her Chairmanship" shall be deleted. Instead the sentence, **"the deputy Commissioner, Dakshina Kannada shall monitor the Sagar Kavach Exercise in the field and co-ordinate with Deputy Commissioner, Udupi Deputy Commissioner, Uttara Kannada, Superintendents of Police of the Coastal Districts, Coastal Security Police including Coast Guard, NMPT, India Navy etc."** shall be included.

By Order and in the name of the Governor of Karnataka,
**PRAKASH Y. K.**
Under Secretary to Government,
Home Department [Law & Order]

**PR - 2148**

## ಇಂಧನ ಸಚಿವಾಲಯ

**ವಿಷಯ :** ಮೆ॥ ಕೃಷ್ಣ ಹೈಡ್ರೊ ಎನರ್ಜಿ ಲಿಮಿಟೆಡ್ ರವರಿಗೆ ಹಂಚಿಕೆಯಾಗಿರುವ 24.75 ಮೆಗಾ ವ್ಯಾಟ್ ಸಾಮರ್ಥ್ಯದ ಗುಂತಗೋಲ ಕಿರು ಜಲ ವಿದ್ಯುತ್ ಯೋಜನೆಯನ್ನು ರದ್ದುಪಡಿಸುವ ಬಗ್ಗೆ.

**ಓದಲಾಗಿದೆ :**
1) ಸರ್ಕಾರಿ ಆದೇಶ ಸಂಖ್ಯೆ : ಇಎನ್ 102 ಎನ್‌ಸಿಇ 2004, ದಿನಾಂಕ : 11–03–2004.
2) ಸರ್ಕಾರಿ ಆದೇಶ ಸಂಖ್ಯೆ : ಇಎನ್ 102 ಎನ್‌ಸಿಇ 2004, ದಿನಾಂಕ : 09–09–2004.
3) ಸರ್ಕಾರಿ ಆದೇಶ ಸಂಖ್ಯೆ : ಇಎನ್ 346 ಎನ್‌ಸಿಇ 2007, ದಿನಾಂಕ : 21–09–2007.
4) ಸರ್ಕಾರಿ ಆದೇಶ ಸಂಖ್ಯೆ : ಇಎನ್ 351 ಎನ್‌ಸಿಇ 2008, (ಬಿ) ದಿನಾಂಕ : 29–10–2009.
5) ದಿನಾಂಕ : 21–12–2011ರಂದು ನಡೆದ ಹಂಚಿಕೆ ಸಮಿತಿಯ ಸಭೆಯ ನಡವಳಿಗಳು.
6) ಕಾರಣ ಕೇಳುವ ನೋಟೀಸ್ ದಿನಾಂಕ : 26–04–2012.
7) ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ, ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ : ಕೆಆರ್ ಇಡಿಎಲ್/06/SH–141/2012–13/2210, ದಿನಾಂಕ : 07/08–08–2012.

**ಪ್ರಸ್ತಾವನೆ :**

ಮೇಲೆ ಓದಲಾದ ಕ್ರಮ ಸಂಖ್ಯೆ (1)ರ ಸರ್ಕಾರಿ ಆದೇಶದಲ್ಲಿ ಮೆ॥ ಜ್ಯೋತಿ ಜಲ ಶಕ್ತಿ ಪ್ರೈವೇಟ್ ಲಿಮಿಟೆಡ್ ಕಂಪೆನಿಗೆ ರಾಯಚೂರು ಜಿಲ್ಲೆಯ, ಲಿಂಗಸಗೂರು ತಾಲ್ಲೂಕಿನ ಗುಂತಗೋಲ ಗ್ರಾಮದ ಬಳಿ ಕೃಷ್ಣ ನದಿಗೆ ಅಡ್ಡಲಾಗಿ 2 ಮೆ.ವ್ಯಾ. ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡಲಾಗಿತ್ತು.

ಮೇಲೆ ಓದಲಾದ ಕ್ರಮ ಸಂಖ್ಯೆ (2)ರ ಸರ್ಕಾರಿ ಆದೇಶದಲ್ಲಿ ಮೆ॥ ಜ್ಯೋತಿ ಜಲ ಶಕ್ತಿ ಪ್ರೈವೇಟ್ ಲಿಮಿಟೆಡ್ ಕಂಪೆನಿಗೆ ರಾಯಚೂರು ಜಿಲ್ಲೆಯ, ಲಿಂಗಸಗೂರು ತಾಲ್ಲೂಕಿನ ಗುಂತಗೋಲ ಗ್ರಾಮದ ಬಳಿ ಹಂಚಿಕೆ ಮಾಡಲಾಗಿದ್ದ ಕಿರು ಜೊ ವಿದ್ಯುತ್ ಯೋಜನೆಯ ಸಾಮರ್ಥ್ಯವನ್ನು 2 ಮೆ.ವ್ಯಾ ನಿಂದ 24.75 ಮೆ.ವ್ಯಾ.ಗೆ ಹೆಚ್ಚಿಸಿ ಆದೇಶಿಸಲಾಗಿತ್ತು.

ಮೇಲೆ ಓದಲಾದ ಕ್ರಮ ಸಂಖ್ಯೆ : (3)ರ ಸರ್ಕಾರಿ ಆದೇಶದಲ್ಲಿ ಮೆ॥ ಜ್ಯೋತಿ ಜಲ ಶಕ್ತಿ ಪ್ರೈವೇಟ್ ಲಿಮಿಟೆಡ್ ಕಂಪೆನಿಯ ಹೆಸರನ್ನು ಮೆ॥ ಗಂಗಾ ಜಲ ಶಕ್ತಿ ಪ್ರೈವೇಟ್ ಲಿಮಿಟೆಡ್ ಎಂದು ಬದಲಾಯಿಸಿ ಆದೇಶಿಸಲಾಗಿತ್ತು.

ಮೇಲೆ ಓದಲಾದ ಕ್ರಮ ಸಂಖ್ಯೆ : (4)ರ ಸರ್ಕಾರಿ ಆದೇಶದಲ್ಲಿ ಮೆ॥ ಗಂಗಾ ಜಲ ಶಕ್ತಿ ಪ್ರೈವೇಟ್ ಲಿಮಿಟೆಡ್ ಕಂಪೆನಿಯ ಹೆಸರನ್ನು ಮೆ॥ ಕೃಷ್ಣ ಹೈಡ್ರೋ ಎನರ್ಜಿ ಲಿಮಿಟೆಡ್ ಎಂದು ಬದಲಾಯಿಸಿ ಆದೇಶಿಸಲಾಗಿತ್ತು.

ಮೇಲೆ ಓದಲಾದ ಕ್ರಮ ಸಂಖ್ಯೆ (5)ರ ದಿನಾಂಕ : 21–12–2012ರಂದು ನಡೆದ ಹಂಚಿಕೆ ಸಮಿತಿ ಸಭೆಯಲ್ಲಿ ಈಗಾಗಲೇ ಕೃಷ್ಣಾ ನದಿಗೆ ಅಡ್ಡಲಾಗಿ ಹಂಚಿಕೆ ಮಾಡಲಾದ ಯೋಜನೆಗಳ ಕುರಿತು ವಿವರವಾಗಿ ಚರ್ಚಿಸಿ ಕೃಷ್ಣಾ ನದಿಗೆ ಅಡ್ಡಲಾಗಿ ಯೋಜನೆ ಹಂಚಿಕೆಯಾಗಿರುವ ಮೆ॥ ಕೃಷ್ಣಾ ಹೈಡ್ರೋ ಎನರ್ಜಿ ಲಿಮಿಟೆಡ್ ರವರು ಯೋಜನೆ ಅನುಷ್ಠಾನದ ನಿಟ್ಟಿನಲ್ಲಿ ಯಾವುದೇ ಪ್ರಗತಿ ತೋರದಿರುವುದರಿಂದ ಸದರಿ ಯೋಜನೆಯನ್ನು ರದ್ದುಪಡಿಸಲು ನೋಟೀಸ್ ನೀಡುವಂತೆ ನಿರ್ಣಯವಾಗಿತ್ತು. ಈ ಹಿನ್ನೆಲೆಯಲ್ಲಿ, ಮೇಲೆ ಓದಲಾದ ಕ್ರಮ ಸಂಖ್ಯೆ : (6)ರ ಕಾರಣ ಕೇಳುವ ನೋಟೀಸಿನಲ್ಲಿ ಯೋಜನೆಯ ಹಂಚಿಕೆ ಆದೇಶವನ್ನು ಏಕೆ ರದ್ದು ಪಡಿಸಬಾರದೆಂದು ಮೆ॥ ಕೃಷ್ಣ ಹೈಡ್ರೋ ಎನರ್ಜಿ ಲಿಮಿಟೆಡ್ ರವರಿಗೆ ನೋಟೀಸನ್ನು ಜಾರಿ ಮಾಡಿ ಸಮಜಾಯಿಷಿಯನ್ನು ನೀಡುವಂತೆ ತಿಳಿಸಲಾಗಿತ್ತು. ಮೆ॥ ಕೃಷ್ಣ ಹೈಡ್ರೋ ಎನರ್ಜಿ ಲಿಮಿಟೆಡ್‌ರವರು ದಿನಾಂಕ : 26–05–2012ರಂದು ಇದಕ್ಕೆ ಉತ್ತರಿಸಿ ಅದೇ ಪ್ರದೇಶದಲ್ಲಿ ತಮ್ಮ ಕಂಪನಿಗೆ ಹಂಚಿಕೆಯಾಗಿರವ 24.75 ಮೆ.ವ್ಯಾ. ಸಾಮರ್ಥ್ಯದ ಬಸವಣ್ಣ ಕಿರು ಜಲ ವಿದ್ಯುತ್ ಯೋಜನೆಯನ್ನು ಅನುಷ್ಠಾನಗೊಳಿಸುವ ಉದ್ದೇಶ ಇಟ್ಟುಕೊಂಡಿರುವುದರಿಂದ ಗುಂತಗೋಲ ಕಿರು ಜಲ ವಿದ್ಯುತ್ ಯೋಜನೆಯ ಪ್ರಗತಿ ಸ್ಥಗಿತಗೊಂಡಿದೆ. ಆದಾಗ್ಯೂ ಸದರಿ ಯೋಜನೆಯನ್ನು ಅನುಷ್ಠಾನಗೊಳಿಸಲು ಅವಶ್ಯವಿರುವ ಇತರ ಇಲಾಖೆಗಳ ಅನುಮೋದನೆಗಳನ್ನು ಹಾಗೂ ಯೋಜನೆಗೆ ಜಮೀನನ್ನು ಪಡೆಯುವ ಪ್ರಕ್ರಿಯೆಗಳು ನಡೆಯುತ್ತಿದೆ ಎಂದು ತಿಳಿಸಿರುತ್ತಾರೆ. ಅಭಿವೃದ್ಧಿದಾರರ ಉತ್ತರವನ್ನು ವ್ಯವಸ್ಥಾಪಕ ನಿರ್ದೇಶಕರು, ಕೆ.ಆರ್.ಇ.ಡಿ.ಎಲ್. ಇವರಿಗೆ ಕಳುಹಿಸಿ ಅವರ ಅಭಿಪ್ರಾಯವನ್ನು ಕೋರಲಾಗಿತ್ತು.

ಮೇಲೆ ಓದಲಾದ ಕ್ರಮ ಸಂಖ್ಯೆ (7)ರ ಪತ್ರದಲ್ಲಿ ವ್ಯವಸ್ಥಾಪಕ ನಿರ್ದೇಶಕರು, ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತರವರು ದಿನಾಂಕ 21–12–2012ರಂದು ನಡೆದ ಹಂಚಿಕೆ ಸಮಿತಿ ನಿರ್ಣಯಿಸಿದಂತೆ ಮುಂದಿನ ಅಗತ್ಯ ಜರುಗಿಸಬಹುದಾಗಿದೆ ಎಂದು ಅಭಿಪ್ರಾಯ ನೀಡಿರುತ್ತಾರೆ.

ಮೆ॥ ಕೃಷ್ಣ ಹೈಡ್ರೋ ಎನರ್ಜಿ ಲಿಮಿಟೆಡ್ ಕಂಪನಿ ರವರಿಗೆ ಯೋಜನೆಯು ಹಂಚಿಕೆಯಾಗಿ 8 ವರ್ಷಗಳು ಕಳೆದರೂ ಯೋಜನೆ ಅನುಷ್ಠಾನದ ನಿಟ್ಟಿನಲ್ಲಿ ಸಮಾದಾನಕರ ಪ್ರಗತಿಯನ್ನು ಸಾಧಿಸಿರುವುದಿಲ್ಲ ಹಾಗೂ ಯೋಜನೆ ಅನುಷ್ಠಾನಗೊಳಿಸಿರುವುದಿಲ್ಲ. ಆದುದರಿಂದ ಹಂಚಕೆ ಆದೇಶವನ್ನು ರದ್ದುಪಡಿಸಲು ತೀರ್ಮಾನಿಸಿ ಈ ಕೆಳಕಂಡಂತೆ ಆದೇಶಿಸಿದೆ :

**ಸರ್ಕಾರಿ ಆದೇಶ ಸಂಖ್ಯೆ : ಇಎನ್ 62 ಎನ್‌ಸಿಇ 2012, ಬೆಂಗಳೂರು, ದಿನಾಂಕ : 01ನೇ ಅಕ್ಟೋಬರ್, 2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳಿಂದಾಗಿ ಸರ್ಕಾರಿ ಆದೇಶ ಸಂಖ್ಯೆ : ಇನ್ 102 ಎನ್‌ಸಿಇ 2004 ದಿನಾಂಕ : 11–03–2004 ಮತ್ತು 09–09–2004ರಲ್ಲಿ ಮೆ॥ ಕೃಷ್ಣ ಹೈಡ್ರೋ ಎನರ್ಜಿ ಲಿಮಿಟೆಡ್ ಕಂಪನಿಗೆ ರಾಯಚೂರು ಜಿಲ್ಲೆಯ, ಲಿಂಗಸಗೂರು ತಾಲ್ಲೂಕಿನ ಗುಂತಗೋಲ ಗ್ರಾಮದ ಬಳೀ ಕೃಷ್ಣ ನದಿಗೆ ಅಡ್ಡಲಾಗಿ ಹಂಚಿಕೆ ಮಾಡಿರುವ 24.75 ಮೆ. ವ್ಯಾ. ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯ ಹಂಚಿಕೆ ಆದೇಶ ಹಾಗೂ ಈ ಸಂಬಂಧ ಸರ್ಕಾರದೊಂದಿಗೆ ಮಾಡಿಕೊಂಡಿಉವ ಒಡಂಬಡಿಕೆಯನ್ನು ತಕ್ಷಣದಿಂದ ಜಾರಿಗೆ ಬರುವಂತೆ ರದ್ದುಪಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೌಸಲ್ಯಾ,**

ಸರ್ಕಾರದ ಅಧೀನ ಕಾರ್ಯದರ್ಶಿ,

ಇಂಧನ ಇಲಾಖೆ

**PR - 2151**

## HORTICULTURE SECRETARIAT

**Sub :** Direct Releases by Government of India for 2012-13-Issue of Adjustment Order for Central share under Centrally Sponsored Scheme on National Horticulture Mission Programme.

**Ref :**
1. Circular No. FD 03 TFP 2012, dated 27-04-2012.
2. Government of India Letter No. F.No. 33-21/2012 – Hort, dated 15-06-2012.
3. Government of India Release Order No. F.No. 18-36/2012 – NHM, dated 06-07-2012.
4. Letter of Director of Horticulture No. ಎಂ.ಡಿ./ಕರಾತೋಮಿಖ/ಸತೋಅ–2/290/L1/2011-12 dated 03-07-2012.
5. Letter of Director of Harticulture No. ಮಿನಿ/ಕರಾತೊಮಿಖ/ವಿನಿ–1/48/2012-13 dated 17-07-2012

**Preamble:**

The Government of India has been transferring substantial funds to the state implementing agencies directly by passing the State budget for implementation of various Centrally Sponsored and Central Plan Schemes. The Comptroller 7 Auditor General in his report on State Finances for the year ending 31st March 2010 has observed that as these funds are not routed through the State Budget, Finance Accounts do not capture the flow of these funds and to that extent the State's receipts and expenditure as well as other fiscal variables/parameters derived from these are understated. The report has suggested that a system should be put in place to ensure proper accounting of these funds and the updated information should thereafter be validated by the State Government as well as the Accountant General (A & E). Public Accounts Committee has also delved on this subject in detail.

2. In view of these observations, the State Government has decided to account for the direct release by the Government of India by incorporating the same as receipts to Consolidated Fund of the State and as expenditure out of Consolidated Fund for onwards release to the State Implementing Agency through its budget for the financial year 2012-13.

3. Now the Director of Horticulture has informed vide letters read at (4) and (5) above that government of India has conveyed the approval for implementation of National Horticulture Mission Programmed (NHM) in the State of Karnataka as read at (2) above during 2012-13 at an outlay of Rs. 14,000 lakhs as per the following details ;

| Total Outlay Approved | GOI share (85%) | State Share (15%) | Project based Activities | Normal Activities |
|---|---|---|---|---|
| 14,000.00 | 11,900.00 | 2,100.00 | 4550.012 | 9449.988 |

4. Further, he has informed that Government of India has released an amount of Rs. 5771.00 lakhs towards Government of India share as read at (3) above and has requested to provide Government Order to carry out necessary adjustment of Government of India share for the financial year 2012-13 in accordance with the Finance Department's Circular read at (1) above.

5. The proposal of the Director of Horticulture has been examined and it is ordered as below :

**GOVERNMENT ORDER NO. HCD 96 HPP 2012, BANGALORE, DATED : 24-07-2012**

Ministry of Agriculture, Department of Agriculture & Co-operation (Horticulture Division), Government of India vide its Government Order cited under reference (3) has made a direct release of **Rs. 5771.00 Lakhs (Rupees Five Thousand Seven Hundred and Seventy One Lakhs Only)** for the financial year 2012-13 for the implementation of Centrally Sponsored Scheme on National Horticulture Mission (NHM) (Nomenclature of the Scheme) towards Government of India share to the "Karnataka State Horticulture Mission Agency, Lalbagh, Bangalore" (Name of Society/Organization). This amount is to be taken as receipt and credited to the Head of Account 1601-03-251-0-46. (As in Col. 7 of Annexure-I of Circular FD 03 TFP 2012 dated 27th April 2012).

2. The entire receipt amount of Rs. 5,771.00 Lakhs (Rupees Five Thousand Seven Hundred and Seventy One Lakhs Only) is to be released onwards to the "Karnataka State Horticulture Mission Agency, Lalbagh, Bangalore" (Name of the Society/Organization) as expenditure for the National Horticulture Mission (Nomenclature of the Scheme) and the same is to be debited to the Head of Account 2401-00-119-4-06. (As in Col. 7 and Row No. 7 of Annexure-I of the Circular of Finance Department No. FD 03 TFP 2012 dated 27th April 2012).

3. The proposed arrangement is for accounting of such direct releases in the State Budget and hence would not entail any net cash outgo from the State's consolidated fund.

4. The Principal Accountant General (A&E) < Karnataka, Bangalore is requested to carry out necessary adjustment as indicated above in the books of accounts for the financial year 2012-13.

5. The Director of Horticulture shall utilize the said funds strictly in accordance with the guidelines issued as per Government of India letters read at (2) and (3) above.

6. This order issues with the concurrence of Internal Financial Advisor, Agriculture and Horticulture Department vide Note No. ತೋಇ 97 ಆಂಆಸ 2012 dated 24-07-2012.

By Order and in the name of the Governor of Karnataka,

**B. C. PRAKASH,**

Under Secretary to Government,

Horticulture Department

**P.R. 2152**

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಬೆಂಗಳೂರು ನಗರ ಜಿಲ್ಲೆ, ಆನೇಕಲ್ ತಾಲ್ಲೂಕು, ಆನೇಕಲ್ ದೊಡ್ಡ ಕೆರೆ ಅಭಿವೃದ್ಧಿ ಕಾಮಗಾರಿಯ ಟೆಂಡರ್ ಅನುಮೋದನೆ ಬಗ್ಗೆ.

**ಓದಲಾಗಿದೆ :** 1. ಸರ್ಕಾರದ ಆದೇಶ ಸಂಖ್ಯೆ: ಸನೀಇ 108 ಮಸಾವಿ 2010, ದಿನಾಂಕ: 28.09.2011.

2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ ಬೆಂಗಳೂರುರವರ ಪತ್ರದ ಸಂಖ್ಯೆ: ಮುಸದ/ ತಾಂ.ಸ.7/ ಸ.ಇಂ.1/ ಬೆಂಗಳೂರು ನಗರ ಜಿ. ಆನೇಕಲ್ ತಾ/ ಆನೇಕಲ್/ ಇ–ಟೆಂಡರ್/ನಂ.3039/ 2011/ 2094, ದಿನಾಂಕ 15.06.2012.

**ಪ್ರಸ್ತಾವನೆ:**

ಮೇಲೆ (1)ರಲ್ಲಿ ಓದಲಾದ ಸರ್ಕಾರದ ಆದೇಶದಲ್ಲಿ 13ನೇ ಹಣಕಾಸು ಆಯೋಗದ ಅನುದಾನದಡಿ ಬೆಂಗಳೂರು ನಗರ ಜಿಲ್ಲೆ, ಆನೇಕಲ್ ತಾಲ್ಲೂಕು, ಆನೇಕಲ್ ದೊಡ್ಡ ಕೆರೆ ಅಭಿವೃದ್ಧಿ ಕಾಮಗಾರಿಯನ್ನು ಕೈಗೊಳ್ಳಲು ಅನುಮೋದನೆ ನೀಡಲಾಗಿದ್ದು. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ ಬೆಂಗಳೂರು ಇವರು ರೂ.180.00ಲಕ್ಷಗಳ ಅಂದಾಜು ಪಟ್ಟಿಗೆ ಆಡಳಿತಾತ್ಮಕ ಅನುಮೋದನೆ ಹಾಗೂ ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬೆಂಗಳೂರು ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ರಾಜ್ಯ ಟೆಂಡರ್ ಬುಲೆಟಿನ್ | 03.03.2012 |
| ಬೆಂಗಳೂರು ನಗರ ಜಿಲ್ಲಾ ಟೆಂಡರ್ ಬುಲೆಟಿನ್ | 03.03.2012 |
| ಕನ್ನಡ ಪ್ರಭ ದಿನಪತ್ರಿಕೆ | 09.03.2012 |

ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಒಬ್ಬರು ಗುತ್ತಿಗೆದಾರರು ಮಾತ್ರ ಭಾಗವಹಿಸಿದ್ದು, ಇವರ ಟೆಂಡರ್ ಅರ್ಹತೆ ಹೊಂದಿದ್ದು, ಇವರ ಆರ್ಥಿಕ ಬಿಡ್ ಅನ್ನು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | | |
|---|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | | ರೂ 155,90,466/– |
| ಪ್ರಸಕ್ತ ಸಾಲಿನ ದರಪಟ್ಟಿಯ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | | ರೂ 159,58,943/– |
| ಕ್ರಮ ಸಂಖ್ಯೆ | ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| 1 | ಎನ್.ಪರಮೇಶ್, 1ನೇ ದರ್ಜೆ ಗುತ್ತಿಗೆದಾರರು | 172,68,260/– | 10.762 ಹೆಚ್ಚು | 8.204 ಹೆಚ್ಚು |

ಮೇಲ್ಕಂಡಂತೆ ಶ್ರೀ ಎನ್.ಪರಮೇಶ್, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಂತೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 8.204 ರಷ್ಟು ಹೆಚ್ಚಾಗಿರುತ್ತದೆ. ಸದರಿ ಟೆಂಡರನ್ನು ಪರಿಶೀಲಿಸಿ ಪರಿಷ್ಕೃತ ದರಗಳ ಮೇಲೆ **ಶೇ.8.00%** ಹೆಚ್ಚಿನ ದರಗಳಿಗೆ ಅಂದರೆ ರೂ.**172,35,658/–** ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 33 ಕೆಜಿದು 2012 (ತಾಂತ್ರಿಕ), ಬೆಂಗಳೂರು, ದಿನಾಂಕ: 11ನೇ ಜುಲೈ 2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬೆಂಗಳೂರು ನಗರ ಜಿಲ್ಲೆ, ಆನೇಕಲ್ ತಾಲ್ಲೂಕು, ಆನೇಕಲ್ ದೊಡ್ಡ ಕೆರೆ ಅಭಿವೃದ್ಧಿ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 159,58,943/–ಗಳ ಮೇಲೆ ಶೇ. 8.00ರಷ್ಟು ಹೆಚ್ಚಿನ ದರದಲ್ಲಿ ಅಂದರೆ ರೂ. 172,35,658/–ಗಳಿಗೆ (ರೂ ಒಂದು ಕೋಟಿ ಎಪ್ಪತ್ತೆರೆಡು ಲಕ್ಷ ಮೂವತ್ತೈದು ಸಾವಿರದ ಆರು ನೂರ ಐವತ್ತೆಂಟು ರೂಪಾಯಿಗಳು ಮಾತ್ರ) ಕಾಮಗಾರಿಯನ್ನು ಶ್ರೀ ಎನ್.ಪರಮೇಶ್, 1ನೇ ದರ್ಜೆ ಗುತ್ತಿಗೆದಾರರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ:20/01/2003ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ರುದ್ರಮೂರ್ತಿ**

PR - 2022

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲ ಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಬೆಳಗಾವಿ ಜಿಲ್ಲೆ, ಹುಕ್ಕೇರಿ ತಾಲ್ಲೂಕಿನ ಕಮತನೂರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಧನ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ಪತ್ರ ಸಂಖ್ಯೆ:ಮುಇಂ/ಸನೀ/ಬಿಜಾಭೂಸ್ವಾಪ್ರ/ 2011–12/1064, ದಿನಾಂಕ 27/02/12.

**ಪ್ರಸ್ತಾವನೆ:**

ಬೆಳಗಾವಿ ಜಿಲ್ಲೆ, ಹುಕ್ಕೇರಿ ತಾಲ್ಲೂಕಿನ ಕಮತನೂರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕಮತನೂರ ಗ್ರಾಮದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸಲು ಅನುದಾನ ಬಿಡುವಂತೆ ಕೋರಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಪ್ರಸ್ತಾವನೆ ಸಲ್ಲಿಸಿದ್ದಾರೆ. ಪ್ರಸ್ತಾಪಿಸಿರುವ ಜಮೀನುಗಳ ಭೂಸ್ವಾಧೀನ ಪ್ರಕ್ರಿಯೆಯ ವಿವರಗಳು ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರ ಅಧಿಸೂಚನೆಯನ್ನು ದಿನಾಂಕ 20/08/92ರಂದು ಹೊರಡಿಸಿದೆ.
- ಭೂಸ್ವಾಧೀನಾಧಿಕಾರಿಗಳು ಐತೀರ್ಪು ರಚಿಸಿದ ದಿನಾಂಕ 28/03/95.

ಭೂಸ್ವಾಧೀನಾಧಿಕಾರಿಗಳು ರಚಿಸಿದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಹುಕ್ಕೇರಿ ಸಿವಿಲ್ ನ್ಯಾಯಾಲಯ(ಹಿರಿಯ ವಿಭಾಗ)ದಲ್ಲಿ ಎಲ್.ಎ.ಸಿ. ಸಂಖ್ಯೆ:95/01ನ್ನು ದಾಖಲಿಸಿದ್ದು, ಸಿವಿಲ್ ನ್ಯಾಯಾಲಯ ದಿನಾಂಕ 09/08/04ರಂದು ನೀಡಿರುವ ಆದೇಶದಲ್ಲಿ ಪ್ರತಿ ಎಕರೆಗೆ ರೂ.1,40,250/–ಗಳ ಬೆಲೆಯನ್ನು ನಿಗದಿಪಡಿಸಿದೆ. ಈ ತೀರ್ಪಿನ ವಿರುದ್ಧ ಸಹಾಯಕ ಆಯುಕ್ತರು, ಬೆಳಗಾವಿ ಇವರು ಕರ್ನಾಟಕ ಉಚ್ಚ ನ್ಯಾಯಾಲಯದ ಸಂಚಾರಿ ಪೀಠ, ಧಾರವಾಡ ಇಲ್ಲಿ ಎಂ.ಎಫ್.ಎ./ಸಿ.ಆರ್.ಓ.179/05ನ್ನು ಸಲ್ಲಿಸಿದ್ದು, ಮಾನ್ಯ ನ್ಯಾಯಾಲಯವು ದಿನಾಂಕ 25/11/10ರಂದು ನೀಡಿದ ತೀರ್ಪಿನಲ್ಲಿ ಪ್ರತಿ ಎಕರೆಗೆ ರೂ.1,70,000/–ಗಳಿಗೆ ಹೆಚ್ಚಿಸಿ ಇತರೆ ಸವಲತ್ತುಗಳೊಂದಿಗೆ ಪಾವತಿಸುವಂತೆ ತೀರ್ಪು ನೀಡಿದೆ. ಈ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯು ಅಭಿಪ್ರಾಯ ಪಟ್ಟಿದೆ. ಈ ಪ್ರಕರಣದಲ್ಲಿ ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ ಸಂ | ಎಲ್‌ಎಸಿ | ಎಂಎಫ್‌ಎ/ ಸಿಆರ್‌ಓಬಿ | ಕಮತನೂರ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 95/01 | 179/05 | 309/6 | 1–18 | 2,20,681–00 |

ಪ್ರಸ್ತಾವನೆಯನ್ನು ಪರಿಶೀಲಿಸಿ, ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 43 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 17ನೇ ಅಕ್ಟೋಬರ್ 2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬೆಳಗಾಂ ಜಿಲ್ಲೆ, ಹುಕ್ಕೇರಿ ತಾಲ್ಲೂಕು ಕಮತನೂರು ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಕಮತನೂರು ಗ್ರಾಮಕ್ಕೆ ಸೇರಿದ ಸರ್ವೆ ನಂಬರ್ 309/6ರ ಒಟ್ಟು 1–18 ಎಕರೆ ಜಮೀನಿಗೆ ಉಚ್ಚ ನ್ಯಾಯಾಲಯದ ತೀರ್ಪಿನಂತೆ ಪರಿಹಾರ ಮೊತ್ತ ರೂ.2,20,681–00ಗಳನ್ನು (ಎರಡು ಲಕ್ಷದ ಇಪ್ಪತ್ತು ಸಾವಿರದ ಆರುನೂರ ಎಂಭತ್ತೊಂದು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು– ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.2,20,681/–ಗಳನ್ನು ಹಂಚಿಕೆ ಮಾಡಿ, ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ,

ಜಲ ಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR - 2174**

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ದುಪ್ಪಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ ಭೂಸ್ವಾಪ್ರ/2012–13/ 2107, ದಿನಾಂಕ 11/04/12.

**ಪ್ರಸ್ತಾವನೆ:**

ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ದುಪ್ಪಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ದುಪ್ಪಳ್ಳಿ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 13/11/97.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 28/08/99.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 11ರಡಿ ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಯಾದಗೀರ್ ಸಿವಿಲ್ ಜಡ್ಜ್(ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ 25/11/2009ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ.52,800/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಪತ್ರ ಸಂಖ್ಯೆ:ಆರ್‌ಡಿ 954 ಎಲ್‌ಸಿಜಿ 2010 ಮತ್ತು ಆರ್‌ಡಿ 963 ಎಲ್‌ಸಿಜಿ 2010, ದಿನಾಂಕ 07/03/10ರಲ್ಲಿ ಅಭಿಪ್ರಾಯ ನೀಡಿದೆ. ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ ಸಂ | ಎಲ್‌ಎಸಿ | ದುಪ್ಪಳ್ಳಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|
| 1 | 9/01 | 318/2ಬಿ | 0–38, 0–02 ಪಿಕೆ | |
| 2 | 10/01 | 318/1ಎ | 0–39, 0–01 ಪಿಕೆ | 788028 |
| | | 315/2 | 2–00 | |
| | | 314/3ಬಿ | 1–39, 0–01 ಪಿಕೆ | |
| | ಒಟ್ಟು | | | **939669** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 68 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 11ನೇ ಸೆಪ್ಟೆಂಬರ್ 2012.**

ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ದುಪ್ಪಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ದುಪ್ಪಳ್ಳಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.9,39,669–00 ಗಳನ್ನು (ಒಂಭತ್ತು ಲಕ್ಷದ ಮೂವತ್ತೊಂಭತ್ತು ಸಾವಿರದ ಆರುನೂರ ಅರವತ್ತೊಂಭತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.

3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.9,39,669/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ.ಸಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ,

ಜಲ ಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR - 2091**

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ಅನೂರ(ಬಿ) ಮತ್ತು ಶಹಾಪೂರ ತಾಲ್ಲೂಕಿನ ಕಂದಳ್ಳಿ ಗ್ರಾಮದ ಭೀಮಾ ನದಿಗೆ ಅಡ್ಡಲಾಗಿ ಕಟ್ಟಿರುವ ಸೇತುವೆಗೆ ಹೋಗುವ ಕೂಡು ರಸ್ತೆಗಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ ಬಿಜಾ/ಭೂಸ್ವಾಪ್ರ/2012–13/ 2727, ದಿನಾಂಕ 11/05/12.

**ಪ್ರಸ್ತಾವನೆ:**

ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ಅನೂರ(ಬಿ) ಮತ್ತು ಶಹಾಪೂರ ತಾಲ್ಲೂಕಿನ ಕಂದಳ್ಳಿ ಗ್ರಾಮದ ಭೀಮಾ ನದಿಗೆ ಅಡ್ಡಲಾಗಿ ಕಟ್ಟಿರುವ ಸೇತುವೆಗೆ ಹೋಗುವ ಕೂಡು ರಸ್ತೆಗಾಗಿ ಸ್ವಾಧೀನಪಡಿಸಿಕೊಂಡ ಅನೂರ(ಬಿ) ಮತ್ತು ಕಂದಳ್ಳಿ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 05/08/2004.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 07/07/2006.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಯಾದಗೀರ್ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿದ್ದು, ಮಾನ್ಯ ನ್ಯಾಯಾಲಯವು ಎಲ್.ಎ.ಸಿ. 3/07, 5/07, 6/07ರಲ್ಲಿ ದಿನಾಂಕ 28/10/09ರಂದು ನೀಡಿದ ಆದೇಶದಲ್ಲಿ ರೂ.1,77,500/–ಗಳನ್ನು ಹಾಗೂ ಎಲ್.ಎ.ಸಿ. 4/07ರಲ್ಲಿ ಪ್ರತಿ ಎಕರೆಗೆ ರೂ.53,250/–ಗಳನ್ನು ನಿಗದಿಪಡಿಸಿದೆ.

ಇನ್ನುಳಿದ ಎಲ್.ಎ.ಸಿ. ಪ್ರಕರಣ ಸಂಖ್ಯೆ:34/07, 35/07, 37/07, 38/07 ಮತ್ತು 39/07ರಲ್ಲಿ ಶೋರಾಪೂರ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯವು ದಿನಾಂಕ 06/12/08ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ.77,007/–ಗಳ ಭೂಮೌಲ್ಯ ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ದಿನಾಂಕ 19/07/10ರಂದು ಅಭಿಪ್ರಾಯ ನೀಡಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ ಸಂ | ಎಲ್‌ಎಸಿ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 3/07 | 204/3 | ಅನೂರು ಬಿ | 0–32 | 366994 |
| 2 | 4/07 | 195/3 | ಅನೂರು ಬಿ | 1–02 | 109282 |
| 3 | 5/07 | 202/3 | ಅನೂರು ಬಿ | 1–18 | 664362 |
| 4 | 6/07 | 201/3 | ಅನೂರು ಬಿ | 0–24 | 275492 |
| 5 | 34/07 | 68/4 | ಕಂದಳ್ಳಿ | 1–18 | 191269 |
| 6 | 35/07 | 85/5 | ಕಂದಳ್ಳಿ | 0–22 | 72614 |

| ಕ್ರ. ಸಂ | ಎಲ್‌ಎಸಿ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 7 | 37/07 | 69/3 | ಕಂದಳ್ಳಿ | 0–17 | 56132 |
| 8 | 38/07 | 71/7 | ಕಂದಳ್ಳಿ | 1–10 | 164900 |
| 9 | 39/07 | 86/7 | ಕಂದಳ್ಳಿ | 0–24 | 79204 |
| | ಒಟ್ಟು | | | | **1980249** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 81 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 11ನೇ ಸೆಪ್ಟೆಂಬರ್ 2012.**

ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ಅನೂರ(ಬಿ) ಮತ್ತು ಶಹಾಪೂರ ತಾಲ್ಲೂಕಿನ ಕಂದಳ್ಳಿ ಗ್ರಾಮದ ಭೀಮಾ ನದಿಗೆ ಅಡ್ಡಲಾಗಿ ಕಟ್ಟಿರುವ ಸೇತುವೆಗೆ ಹೋಗುವ ಕೂಡು ರಸ್ತೆಗಾಗಿ ಸ್ವಾಧೀನಪಡಿಸಿಕೊಂಡ ಅನೂರ(ಬಿ) ಮತ್ತು ಕಂದಳ್ಳಿ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.19,80,249–00ಗಳನ್ನು (ಹತ್ತೊಂಭತ್ತು ಲಕ್ಷದ ಎಂಭತ್ತು ಸಾವಿರದ ಇನ್ನೂರ ನಲವತ್ತೊಂಭತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು– ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.19,80,249/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ.ಸಿ. ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ,
ಜಲ ಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR - 2092**

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಕೊಪ್ಪಳ ಜಿಲ್ಲೆ ಮತ್ತು ತಾಲ್ಲೂಕಿನ ದನಗಲದೊಡ್ಡಿ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 23/08/12ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ ಬಿಜೆಪಿ/ಭೂಸ್ವಾಪ್ರ/2012–13/4724.

**ಪ್ರಸ್ತಾವನೆ:**

ಕೊಪ್ಪಳ ಜಿಲ್ಲೆ ಮತ್ತು ತಾಲ್ಲೂಕಿನ ದನಗಲದೊಡ್ಡಿ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ದನಗಲದೊಡ್ಡಿ ಗ್ರಾಮದ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಪ್ರಕರಣಗಳಲ್ಲಿ ಮಾನ್ಯ ನ್ಯಾಯಾಲಯವು ನೀಡಿದ ತೀರ್ಪಿನಂತೆ ಹೆಚ್ಚಿನ ಪರಿಹಾರ ಧನ ಪಾವತಿಸಲು ರೂ.15,18,376–00ಗಳನ್ನು ಬಿಡುಗಡೆ ಮಾಡುವಂತೆ ಕೋರಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ಪತ್ರದಲ್ಲಿ ಪ್ರಸ್ತಾವನೆ ಸಲ್ಲಿಸಿದ್ದಾರೆ. ಭೂಸ್ವಾಧೀನ ಪ್ರಕ್ರಿಯೆಯ ವಿವರಗಳು ಕೆಳಕಂಡಂತಿವೆ:

- ಭೂಸ್ವಾಧೀನ ಕಾಯ್ದೆ ಕಲಂ 4(1)ರ ಅಧಿಸೂಚನೆ ದಿನಾಂಕ 19/02/09.
- ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ರಚಿಸಿದ ದಿನಾಂಕ 31/03/11

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದ ಭೂಮಾಲೀಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿ ನ್ಯಾಯಾಲಯದಿಂದ ಹೆಚ್ಚಿನ ಪರಿಹಾರ ಧನಕ್ಕೆ ಆದೇಶ ಪಡೆದುಕೊಂಡಿದೆ. ನ್ಯಾಯಾಲಯದ ತೀರ್ಪಿನಲ್ಲಿ ಭೂಸ್ವಾಧೀನಾಧಿಕಾರಿಗಳು ಪ್ರತಿ ಎಕರೆಗೆ ನಿಗದಿಪಡಿಸಿದ್ದ ರೂ.30,050/–ಗಳಿಂದ ಪ್ರತಿ ಎಕರೆಗೆ ರೂ.1,80,000/–ಗಳಂತೆ ಹೆಚ್ಚಿಸಿ ಶಾಸನಬದ್ಧ ಇತರೆ ಸವಲತ್ತುಗಳನ್ನು ನೀಡಲು ಆದೇಶಿಸಲಾಗಿದೆ.

ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆ ಕಾನೂನು ಕೋಶವು ಪತ್ರ ಸಂಖ್ಯೆ:ಆರ್‌ಡಿ 69 ಎಲ್‌ಸಿಜಿ 2012, ದಿನಾಂಕ 05/07/12ರಲ್ಲಿ ನಿರ್ಧಾರ ಕೈಗೊಂಡಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್‌ಎಸಿ ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 35/11 | 7/ಅ/2/1 | ದನಗಲದೊಡ್ಡಿ | 2–15 | 801337 |
| 2 | 36/11 | 7/ಅ2 | ದನಗಲದೊಡ್ಡಿ | 2–05 | 717039 |
| | ಒಟ್ಟು | | | | 1518376 |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 121 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 25ನೇ ಸೆಪ್ಟೆಂಬರ್ 2012.**

ಕೊಪ್ಪಳ ಜಿಲ್ಲೆ ಮತ್ತು ತಾಲ್ಲೂಕಿನ ದನಗಲದೊಡ್ಡಿ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ದನಗಲದೊಡ್ಡಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಕೊಪ್ಪಳ (ಹಿರಿಯ ಶ್ರೇಣಿ) ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.15,18,376/–ಗಳನ್ನು (ಹದಿನೈದು ಲಕ್ಷದ ಹದಿನೆಂಟು ಸಾವಿರದ ಮುನ್ನೂರ ಎಪ್ಪತ್ತಾರು ರೂ.ಗಳು ಮಾತ್ರ) ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ರೂ.15,18,376/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ.ಸಿ.ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ,

ಜಲ ಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR - 2162**

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಕೊಪ್ಪಳ ಜಿಲ್ಲೆ ಮತ್ತು ತಾಲ್ಲೂಕಿನ ಬೂದುಗುಂಪಾ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ

**ಓದಲಾಗಿದೆ:** ಮುಖ್ಯ ಇಂಜನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 29/08/12ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ ಬಿಜೆಪಿ/ಭೂಸ್ವಾಪ್ರ/2012–13/4893.

**ಪ್ರಸ್ತಾವನೆ:**

ಕೊಪ್ಪಳ ಜಿಲ್ಲೆ ಮತ್ತು ತಾಲ್ಲೂಕಿನ ಬೂದುಗುಂಪಾ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಬೂದುಗುಂಪಾ ಗ್ರಾಮದ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಪ್ರಕರಣಗಳಲ್ಲಿ ಮಾನ್ಯ ನ್ಯಾಯಾಲಯವು ನೀಡಿದ ತೀರ್ಪಿನಂತೆ ಹೆಚ್ಚಿನ ಪರಿಹಾರ ಧನ ಪಾವತಿಸಲು ರೂ.44,81,946–00ಗಳನ್ನು ಬಿಡುಗಡೆ ಮಾಡುವಂತೆ ಕೋರಿ ಮುಖ್ಯ ಇಂಜನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ಪತ್ರದಲ್ಲಿ ಪ್ರಸ್ತಾವನೆ ಸಲ್ಲಿಸಿದ್ದಾರೆ. ಭೂಸ್ವಾಧೀನ ಪ್ರಕ್ರಿಯೆಯ ವಿವರಗಳು ಕೆಳಕಂಡಂತಿವೆ:

- ಭೂಸ್ವಾಧೀನ ಕಾಯ್ದೆ ಕಲಂ 4(1)ರ ಅಧಿಸೂಚನೆ ದಿನಾಂಕ 18/09/08.
- ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ರಚಿಸಿದ ದಿನಾಂಕ 31/03/11

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದ ಭೂಮಾಲೀಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿ ನ್ಯಾಯಾಲಯದಿಂದ ಹೆಚ್ಚಿನ ಪರಿಹಾರ ಧನಕ್ಕೆ ಆದೇಶ ಪಡೆದುಕೊಂಡಿದೆ. ನ್ಯಾಯಾಲಯದ ತೀರ್ಪಿನಲ್ಲಿ ಭೂಸ್ವಾಧೀನಾಧಿಕಾರಿಗಳು ಪ್ರತಿ ಎಕರೆಗೆ ನಿಗದಿಪಡಿಸಿದ್ದ ರೂ.29,100/–ಗಳಿಂದ ಪ್ರತಿ ಎಕರೆಗೆ ರೂ.1,80,000/–ಗಳಂತೆ ಹೆಚ್ಚಿಸಿ ಶಾಸನಬದ್ದ ಇತರೆ ಸವಲತ್ತುಗಳನ್ನು ನೀಡಲು ಆದೇಶಿಸಲಾಗಿದೆ.

ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆ ಕಾನೂನು ಕೋಶವು ಪತ್ರ ಸಂಖ್ಯೆ:ಆರ್‌ಡಿ 68 ಎಲ್‌ಸಿಜಿ 2012, ದಿನಾಂಕ 05/07/12ರಲ್ಲಿ ನಿರ್ಧಾರ ಕೈಗೊಂಡಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ ಸಂ | ಎಲ್‌ಎಸಿ ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 31/11 | 12/3 | ಬಿಳೆಭಾವಿ | 4–30 | 1737622 |
| 2 | 32/11 | 13/ಆ | ಬಿಳೆಭಾವಿ | 2–06 | 786777 |
| 3 | 33/11 | 12/2 | ಬಿಳೆಭಾವಿ | 4–30 | 1737622 |
| 4 | 34/11 | 8/ಅ | ಬಿಳೆಭಾವಿ | 0–24 | 219925 |
| | ಒಟ್ಟು | | | | **4481946** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 124 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 25ನೇ ಸೆಪ್ಟೆಂಬರ್ 2012.**

ಕೊಪ್ಪಳ ಜಿಲ್ಲೆ ಮತ್ತು ತಾಲ್ಲೂಕಿನ ಬೂದುಗುಂಪಾ ಜಿನುಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಬೂದುಗುಂಪಾ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಕೊಪ್ಪಳ (ಹಿರಿಯ ಶ್ರೇಣಿ) ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.44,81,946/–ಗಳನ್ನು(ನಲವತ್ತಾನ್ಲುಕ್ಕು ಲಕ್ಷದ ಎಂಭತ್ತೊಂದು ಸಾವಿರದ ಒಂಭೈನೂರ ನಲವತ್ತಾರು ರೂ.ಗಳು ಮಾತ್ರ) ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು– ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ರೂ.44,81,946/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ.ಪಿ. ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ,

ಜಲ ಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR - 2161**

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಬೀದರ್ ಜಿಲ್ಲೆ ಮತ್ತು ತಾಲ್ಲೂಕಿನ ಅಷ್ಟೂರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:**

1. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರಸಂಖ್ಯೆ:ಮುಇಂ/ಸನೀ(ಉ)ವ/ ಬಿಜಾ/ಭೂಸ್ವಾಪ್ರ/2012–13/4578, ದಿನಾಂಕ 10/08/12.
2. ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಿಭಾಗ, ಬೀದರ್ ಇವರ ಪತ್ರ ಸಂಖ್ಯೆ:ಕಾನೀ/ಸನೀವಿ/ ಬೀದರ್/ಡಿಎಂ/ಮಿರ್ಜಾಪೂರ(ಟಿ)/ಇಪಿಪ್ರ/2012–13/2432, ದಿನಾಂಕ 18/09/12.

**ಪ್ರಸ್ತಾವನೆ:**

ಬೀದರ್ ಜಿಲ್ಲೆ ಮತ್ತು ತಾಲ್ಲೂಕಿನ ಅಷ್ಟೂರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಮಿರ್ಜಾಪೂರ(ಟಿ) ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಧನ ರೂ.35,91,562/–ಗಳ ಶೇ.50ರಷ್ಟು ರೂ.17,95,781/–ಗಳನ್ನು ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (1)ರಲ್ಲಿ ಓದಲಾದ ಪತ್ರದಲ್ಲಿ ಪ್ರಸ್ತಾವನೆ ಸಲ್ಲಿಸಿದ್ದಾರೆ. ಭೂಸ್ವಾಧೀನ ಪ್ರಕ್ರಿಯೆ ವಿವರಗಳು ಕೆಳಕಂಡಂತಿದೆ.

- ಭೂಸ್ವಾಧೀನ ಕಾಯ್ದೆ ಕಲಂ 4(1)ರ ಅಧಿಸೂಚನೆಯನ್ನು ದಿನಾಂಕ 27/01/05 ರಂದು ಹೊರಡಿಸಲಾಗಿದೆ.
- ಭೂಸ್ವಾಧೀನಾಧಿಕಾರಿಗಳು ಐತೀರ್ಪು ರಚಿಸಿದ ದಿನಾಂಕ 29/02/08

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಬೀದರ್ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ:6/09ನ್ನು ದಾಖಲಿಸಿದ್ದು, ಮಾನ್ಯ ನ್ಯಾಯಾಲಯವು ದಿನಾಂಕ 18/12/10ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ.8,24,010/–ಗಳನ್ನು ನಿಗದಿಪಡಿಸಿ ಇತರೆ ಸವಲತ್ತುಗಳೊಂದಿಗೆ ಪಾವತಿಸುವಂತೆ ಆದೇಶಿಸಿದೆ. ಈ ಆದೇಶದ ವಿರುದ್ಧ ಉಚ್ಚ ನ್ಯಾಯಾಲಯದಲ್ಲಿ ಮೇಲ್ಮನವಿ ಸಲ್ಲಿಸಲು ಕಂದಾಯ ಇಲಾಖೆ ಕಾನೂನು ಅಧಿಕಾರಿ–3, ಕಂದಾಯ ಇಲಾಖೆ(ಎಲ್ಎಸಿ) ಇವರು ದಿನಾಂಕ 31/07/12ರ ಪತ್ರದಲ್ಲಿ ಅಭಿಪ್ರಾಯ ಪಟ್ಟಿರುತ್ತಾರೆ. ಆದರೆ, ಸದರಿ ಪ್ರಕರಣಕ್ಕೆ ಸಂಬಂಧಿಸಿದಂತೆ ಮಾನ್ಯ ಪ್ರಿನ್ಸಿಪಲ್ ಸಿವಿಲ್ ಜಡ್ಜ್ ನ್ಯಾಯಾಲಯ, ಬೀದರ್ ಇವರು ಬೀದರ್ ಸಣ್ಣ ನೀರಾವರಿ ವಿಭಾಗದ ಕಾರ್ಯಪಾಲಕ ಇಂಜಿನಿಯರ್‌ರವರಿಗೆ ಅರೆಸ್ಟ್ ವಾರೆಂಟ್ ಜಾರಿಗೊಳಿಸಲಾಗುವುದೆಂದು ನೋಟೀಸ್ ಜಾರಿ ಮಾಡಿರುವುದರಿಂದ, ಪರಿಹಾರ ಮೊತ್ತದ ಶೇ.50ರಷ್ಟು ಮೊತ್ತವನ್ನು ಬಿಡುಗಡೆ ಮಾಡಬೇಕೆಂದು ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಿಭಾಗ, ಬೀದರ್ ಇವರು ಮೇಲೆ (2)ರಲ್ಲಿ ಓದಲಾದ ಪತ್ರದಲ್ಲಿ ಕೋರಿದ್ದಾರೆ.

ಪ್ರಸ್ತಾವನೆಯನ್ನು ಪರಿಶೀಲಿಸಿ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 125 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 12ನೇ ಅಕ್ಟೋಬರ್ 2012.**

ಬೀದರ್ ಜಿಲ್ಲೆ ಮತ್ತು ತಾಲ್ಲೂಕಿನ ಅಷ್ಟೂರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಮಿರ್ಜಾಪೂರ(ಟಿ) ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಪರಿಹಾರ ಮೊತ್ತದ ಶೇ.50ರಷ್ಟು ಅಂದರೆ ರೂ.17,95,781–00ಗಳನ್ನು (ಹದಿನೇಳು ಲಕ್ಷದ ತೊಂಭತ್ತೈದು ಸಾವಿರದ ಏಳುನೂರ ಎಂಭತ್ತೊಂದು ರೂ.ಗಳು ಮಾತ್ರ) **ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಿಭಾಗ, ಬೀದರ್ ಇವರಿಗೆ ಒದಗಿಸಿರುವ ಅನುದಾನದಲ್ಲಿ ಸೂಕ್ತ ಲೆಕ್ಕ ಶೀರ್ಷಿಕೆಯಡಿ ಪಾವತಿಸಲು** ಹಾಗೂ ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಸರ್ಕಾರವು ಅನುಮೋದನೆ ನೀಡಿದೆ.

1. ಸಿವಿಲ್ ನ್ಯಾಯಾಲಯದ ಆದೇಶದ ವಿರುದ್ಧ ಉಚ್ಚ ನ್ಯಾಯಾಲಯದಲ್ಲಿ ಮೇಲ್ಮನವಿ ಸಲ್ಲಿಸಲು ಕ್ರಮ ಕೈಗೊಳ್ಳುವುದು.
2. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
3. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
4. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕ ಪ್ರತ್ಯಾಯೋಜನೆ ಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ,
ಜಲ ಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR - 2168**

**ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ**

**ತಿದ್ದುಪಡಿ ಆದೇಶ**

**ಸಂಖ್ಯೆ: ಸಿಆಸುಇ 230 ಸಅಸೇ 2012 ಬೆಂಗಳೂರು, ದಿನಾಂಕ: 11.10.2012**

ಸರ್ಕಾರದ ಅಧಿಸೂಚನೆ ಸಂಖ್ಯೆ: ಸಿಆಸುಇ 230 ಸಅಸೇ 2012 ದಿನಾಂಕ: 06–08–2012 4ನೇ ಸಾಲಿನಲ್ಲಿ **"ಜಂಟಿ ನಿರ್ದೇಶಕರು (ಯೋಜನೆ), ನಗರಾಭಿವೃದ್ಧಿ ಇಲಾಖೆ"** ಎಂಬುದನ್ನು **"ಜಂಟಿ ನಿರ್ದೇಶಕರು (ಯೋಜನೆ), ವಸತಿ ಮತ್ತು ನಗರಾಭಿವೃದ್ಧಿ ಇಲಾಖೆ"** ಎಂದು ತಿದ್ದಿ ಓದಿಕೊಳ್ಳತಕ್ಕದ್ದು ಉಳಿದಂತೆ ಯಾವುದೇ ಬದಲಾವಣೆ ಇರುವುದಿಲ್ಲ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಹೆಚ್. ಕೆ. ಲಕ್ಷ್ಮೀನಾರಾಯಣ ರಾವ್**
ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಆಸುಇ (ಸೇವೆಗಳು–3)

**PR - 2172**